ಟೆಂಡರಿಗಿಡಲಾದ ಮೊತ್ತ ರೂ.1,29,31,943–00ಗಳ ಮೇಲೆ ಶೇಕಡ 12.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ.1,44,83,776–00ಗಳಿಗೆ ಕಾಮಗಾರಿಯನ್ನು ಶ್ರೀ ಜಿ.ಓ. ರಾಜು, 1ನೇ ದರ್ಜೆ ಗುತ್ತಿಗೆದಾರರು, ದಾವಣಗೆರೆ ಇವರಿಗೆ ವಹಿಸಲು ಸಭೆಯಲ್ಲಿ ತೀರ್ಮಾನಿಸಿದ್ದು, ಇದಕ್ಕೆ ಗುತ್ತಿಗೆದಾರರು ಸಮ್ಮತಿ ನೀಡಿರುವುದಾಗಿ ತಿಳಿಸಿ ಸಭೆಯ ನಡವಳಿಗಳೊಂದಿಗೆ ಸದರಿಯವರ ಟೆಂಡರ್‌ನ್ನು ಅಂಗೀಕರಿಸಲು ಮೇಲೆ (2)ರಲ್ಲಿ ಓದಲಾದ ಪತ್ರದಲ್ಲಿ ಅಧ್ಯಕ್ಷರು, ಟೆಂಡರ್ ಪರಿಶೀಲನಾ ಸಮಿತಿ, ಸಣ್ಣ ನೀರಾವರಿ ಇಲಾಖೆ ಹಾಗೂ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ಇವರು ಶಿಫಾರಸ್ಸು ಮಾಡಿರುತ್ತಾರೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 68 ಕೆಜಿದು 2008, ಬೆಂಗಳೂರು, ದಿನಾಂಕ 24ನೇ ಡಿಸೆಂಬರ್ 2008.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಚಿತ್ರದುರ್ಗ ಜಿಲ್ಲೆ, ಚಿತ್ರದುರ್ಗ ತಾಲ್ಲೂಕು, ಕಲ್ಲಹಳ್ಳಿ ಕೆರೆ ಅಭಿವೃದ್ಧಿ ಕಾಮಗಾರಿಯ ಮಂಜೂರಾದ ಅಂದಾಜು ಪಟ್ಟಿ ಹಾಗೂ ಪ್ರಸಕ್ತ ಸಾಲಿನ ದರಪಟ್ಟಿಯಂತೆ ಪರಿಷ್ಕರಿಸಿದ ಟೆಂಡರಿಗೆ ಇಡಲಾದ ಮೊತ್ತ ರೂ.1,29,31,943–00ಗಳ ಮೇಲೆ ಶೇಕಡ 12.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ.1,44,83,776–00ಗಳಿಗೆ (ಒಂದು ಕೋಟಿ ನಲವತ್ತಾಲ್ಕು ಲಕ್ಷದ ಎಂಭತ್ಮೂರು ಸಾವಿರದ ಏಳುನೂರ ಎಪ್ಪತ್ತಾರು ರೂ.ಗಳು ಮಾತ್ರ) ಶ್ರೀ ಜಿ.ಓ. ರಾಜು, 1ನೇ ದರ್ಜೆ ಗುತ್ತಿಗೆದಾರರು, ದಾವಣಗೆರೆ ಇವರಿಗೆ ಕಾಮಗಾರಿಯನ್ನು ಕೆಳಕಂಡ ಷರತ್ತುಗಳೊಂದಿಗೆ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗದಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.
3. ಅಂಗೀಕರಿಸಿದ ಮೇಲ್ಕಂಡ ಮೊತ್ತಕ್ಕಿಂತ ಹೆಚ್ಚುವರಿಯಾಗಿ ಯಾವುದೇ ಕ್ಲೇಮುಗಳನ್ನು ಸರ್ಕಾರವು ಪರಿಗಣಿಸುವುದಿಲ್ಲ.
4. ಅಸಹಜ ದರಗಳನ್ನು ಸಮನ್ವಯಪಡಿಸಿಕೊಳ್ಳುವುದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 01 ಟಿಎಫ್‌ಪಿ 2002, ದಿನಾಂಕ: 20/01/2003ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 152

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲ ಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ಬಿಜಾಪುರ ಜಿಲ್ಲೆ, ಇಂಡಿ ತಾಲ್ಲೂಕು ಇಂಚಗೇರಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 22/11/2008ರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/ 2008–09/6168.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಬಿಜಾಪುರ ಜಿಲ್ಲೆ, ಇಂಡಿ ತಾಲ್ಲೂಕು ಇಂಚಗೇರಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಇಂಚಗೇರಿ ಗ್ರಾಮದ ಜಮೀನುಗಳಿಗೆ ಬಿಜಾಪುರ 2ನೇ ಹೆಚ್ಚುವರಿ (ಹಿರಿಯ ಶ್ರೇಣಿ) ನ್ಯಾಯಾಧೀಶರು ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

– ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 25/05/2000
– ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 07/03/2003.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಬಿಜಾಪುರ 2ನೇ ಹೆಚ್ಚುವರಿ (ಹಿರಿಯ ಶ್ರೇಣಿ) ನ್ಯಾಯಾಧೀಶರು ಭೂಸ್ವಾಧೀನ ಪ್ರಕರಣಗಳನ್ನು ದಾಖಲಿಸಿದ್ದು, ಈ ಪ್ರಕರಣಗಳಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ.

ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯು ಪತ್ರ ಸಂಖ್ಯೆ:ಲಾ 2397 ಎಲ್‌ಬಿಎಸ್ 2005, ದಿನಾಂಕ 10/02/06 ಹಾಗೂ ಲಾ 2398 ಎಲ್‌ಬಿಎಸ್ 2005, ದಿನಾಂಕ 10/02/06ರಲ್ಲಿ

ಅಭಿಪ್ರಾಯ ನೀಡಿದೆ. ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್‌ಎಸಿ ಸಂಖ್ಯೆ. | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 188/03 | 432/1 | ಇಂಚಗೇರಿ | 3–32 | 219268 |
| 2 | 187/03 | 429 | ಇಂಚಗೇರಿ | 4–35 | 275882 |
| | | | | **ಒಟ್ಟು** | **495150** |

* ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 138 ಭೂಸ್ವಾಪ್ರ 2007(ಭಾ), ಬೆಂಗಳೂರು, ದಿನಾಂಕ 24ನೇ ಡಿಸೆಂಬರ್ 2008.**

ಬಿಜಾಪುರ ಜಿಲ್ಲೆ, ಇಂಡಿ ತಾಲ್ಲೂಕಿನ ಇಂಚಗೇರಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಇಂಚಗೇರಿ ಗ್ರಾಮಕ್ಕೆ ಸೇರಿದ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.4,95,150–00ಗಳನ್ನು (ನಾಲ್ಕು ಲಕ್ಷದ ತೊಂಭತ್ತೈದು ಸಾವಿರದ ನೂರ ಐವತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2008–09ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂ:ಎಫ್‌ಡಿ 21 ಟಿಎಫ್‌ಪಿ 2006 ದಿನಾಂಕ 02/09/2006ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 153

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ಹಾವೇರಿ ಜಿಲ್ಲೆ, ಬ್ಯಾಡಗಿ ತಾಲ್ಲೂಕಿನ ಅಂಗಾರಗಟ್ಟಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮಾಸಣಗಿ ಮತ್ತು ಹಿರೇನಂದಿಹಳ್ಳಿ ಗ್ರಾಮಗಳ ಜಮೀನುಗಳಿಗೆ ಮಾನ್ಯ ಸರ್ವೋಚ್ಚ ನ್ಯಾಯಾಲಯದ ತೀರ್ಪಿನಂತೆ ಭೂ ಬಾಡಿಗೆ ಅಥವಾ ಬೆಳೆ ನಷ್ಟ ಪರಿಹಾರ ಸಂದಾಯ ಮಾಡುವ ಬಗ್ಗೆ.

**ಓದಲಾಗಿದೆ:**
1. ದಿನಾಂಕ 06/10/08ರ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ ಭೂಸ್ವಾಪ್ರ/08–09/5439.
2. ದಿನಾಂಕ 10/02/2006ರ ಸರ್ಕಾರಿ ಪತ್ರ ಸಂಖ್ಯೆ:ಸನೀಇ 44 ಭೂಸ್ವಾಪ್ರ 2001.

**ಪ್ರಸ್ತಾವನೆ:**

ಹಾವೇರಿ ಜಿಲ್ಲೆ, ಬ್ಯಾಡಗಿ ತಾಲ್ಲೂಕಿನ ಅಂಗಾರಗಟ್ಟಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮಾಸಣಗಿ ಮತ್ತು ಹಿರೇನಂದಿಹಳ್ಳಿ ಗ್ರಾಮಗಳ ಜಮೀನುಗಳಿಗೆ ಹೆಚ್ಚುವರಿ ಪರಿಹಾರನ ಧನವನ್ನು ಸಂದಾಯ ಮಾಡುವ ಬಗ್ಗೆ ಮಾನ್ಯ ಉಚ್ಚ ನ್ಯಾಯಾಲಯದಲ್ಲಿ ದಾಖಲಿಸಲಾಗಿದ್ದ ರಿಟ್ ಅರ್ಜಿ ಸಂಖ್ಯೆ:3121–3140/2001 ಹಾಗೂ 33367/2001ರಲ್ಲಿ ದಿನಾಂಕ 29/05/02ರಂದು ನೀಡಿರುವ ತೀರ್ಪಿನಲ್ಲಿ ಸ್ವಾಧೀನಪಡಿಸಿಕೊಂಡ ಜಮೀನಿನ ಕಬ್ಜೆಯನ್ನು ಪಡೆದ ಕ್ರಮವಾಗಿ ಹಿರೇನಂದಿಹಳ್ಳಿ ಗ್ರಾಮದ ಜಮೀನುಗಳಿಗೆ ದಿನಾಂಕ 12/08/1968 ಮತ್ತು ಮಾಸಣಗಿ ಗ್ರಾಮದ ಜಮೀನುಗಳಿಗೆ ದಿನಾಂಕ 22/10/1970ರಿಂದ ಪಾವತಿಸಲು ಆದೇಶಿಸಲಾಗಿದೆ. ಕಬ್ಜೆ ಪಡೆದ ದಿನಾಂಕದಿಂದ ಬಡ್ಡಿ ಪಾವತಿಸುವ ವಿಷಯದಲ್ಲಿ ಉಚ್ಚ ನ್ಯಾಯಾಲಯದ ತೀರ್ಪನ್ನು ಉಲ್ಲೇಖಿಸಿ ಮಾನ್ಯ ಸರ್ವೋಚ್ಚ ನ್ಯಾಯಾಲಯದಲ್ಲಿ ದಾಖಲಿಸಲಾಗಿದ್ದ ಎಸ್.ಎಲ್.ಪಿ. ಸಂಖ್ಯೆ:15590–15610/03–ಸಿವಿಲ್ ಅಪೀಲ್ ಸಂಖ್ಯೆ: 819–839/05 ಸರ್ಕಾರದ ಪರವಾಗಿ ತೀರ್ಪು ಆಗಿದ್ದು, ಕಬ್ಜೆ ಪಡೆದ ದಿನಾಂಕದಿಂದ ನೀಡಲಾಗಿದ್ದ 4(1)ರ ಅಧಿಸೂಚನೆಯ ದಿನಾಂಕದಿಂದ ಲೆಕ್ಕ ಹಾಕಿ ನ್ಯಾಯಾಲಯದಲ್ಲಿ ಠೇವಣಿ ಇಡಲಾಗಿದ್ದ ಮೊತ್ತವನ್ನು ಮೇಲೆ (2)ರಲ್ಲಿ ಓದಲಾದ ದಿನಾಂಕ 10/02/06ರ ಪತ್ರದಲ್ಲಿ ಹಿಂಪಡೆಯಲು ಸೂಚಿಸಲಾಗಿದೆ. ಮಾನ್ಯ ಸರ್ವೋಚ್ಚ ನ್ಯಾಯಾಲಯದ ತೀರ್ಪಿನಲ್ಲಿ 4(1)ರ ಅಧಿಸೂಚನೆಯ ಹಿಂದಿನ ಅವಧಿಗೆ ಭೂ ಬಾಡಿಗೆ ಅಥವಾ ನಷ್ಟ ಪರಿಹಾರವನ್ನು ಪಡೆಯಲು

ಪ್ರತಿವಾದಿಗಳು ತಮ್ಮ ಕ್ಲೇಮ್‌ನ್ನು ಸಲ್ಲಿಸಲು ಸ್ವತಂತ್ರರೆಂದು ತಿಳಿಸಿತ್ತು. ಈ ವಿಚಾರದಲ್ಲಿ ಪ್ರತಿವಾದಿಗಳಾದ ಭೂಮಾಲೀಕರು ಸಂಬಂಧಪಟ್ಟ ಭೂಸ್ವಾಧೀನಾಧಿಕಾರಿಗಳಲ್ಲಿ ಅರ್ಜಿ ಸಲ್ಲಿಸಿ ನಂತರ ಉಚ್ಚ ನ್ಯಾಯಾಲಯದಲ್ಲಿ ಸಹ ಈ ವಿಷಯದಲ್ಲಿ ರಿಟ್ ಅರ್ಜಿ ಸಂಖ್ಯೆ:3361/07ನ್ನು ದಾಖಲಿಸಿ ಇದರಲ್ಲಿ ಮಾನ್ಯ ನ್ಯಾಯಾಲಯದಲ್ಲಿ ದಿನಾಂಕ 03/04/07ರಲ್ಲಿ ನೀಡಿದ ತೀರ್ಪಿನಲ್ಲಿ ಅರ್ಜಿದಾರರಿಗೆ 4(1)ರ ಪೂರ್ವಾವಧಿಗೆ ನಷ್ಟ ಪರಿಹಾರವನ್ನು ನೀಡಲು ಆದೇಶ ನೀಡಿದೆ.

ಮಾನ್ಯ ಉಚ್ಚ ನ್ಯಾಯಾಲಯದ ಆದೇಶದ ಜಾರಿಗಾಗಿ ಉಪ ವಿಭಾಗಾಧಿಕಾರಿಗಳು, ಹಾವೇರಿ ಇವರು ಭೂಮಾಲೀಕರಿಗೆ ಪಾವತಿಸಬೇಕಾದ ಭೂಬಾಡಿಗೆ ಅಥವಾ ಬೆಳೆ ನಷ್ಟ ಪರಿಹಾರ ನಿಗದಿಪಡಿಸಿ ದಿನಾಂಕ 23/07/08ರಲ್ಲಿ ಐತೀರ್ಪು ಹೊರಡಿಸಿದ್ದು ನಂತರ ಈ ಐತೀರ್ಪಿಗೆ ದಿನಾಂಕ 13/08/08ರಂದು ಹೊರಡಿಸಲಾದ ತಿದ್ದುಪಡಿ ಆದೇಶದಂತೆ ಒಟ್ಟು ರೂ.38,36,381–00ಗಳನ್ನು ಭೂಮಾಲೀಕರಿಗೆ ನಷ್ಟ ಪರಿಹಾರವನ್ನು ಪಾವತಿಸಲು ಮೇಲೆ (1)ರಲ್ಲಿ ಓದಲಾದ ದಿನಾಂಕ 06/10/08ರ ಪತ್ರದಲ್ಲಿ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್‌ರವರು ಸರ್ಕಾರಕ್ಕೆ ಪ್ರಸ್ತಾವನೆಯನ್ನು ಸಲ್ಲಿಸಿರುತ್ತಾರೆ.

ಪ್ರಸ್ತಾವನೆಯನ್ನು ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 130 ಭೂಸ್ವಾಪ್ರ 2008, ಬೆಂಗಳೂರು, ದಿನಾಂಕ 24ನೇ ಡಿಸೆಂಬರ್ 2008.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಮಾನ್ಯ ಉಚ್ಚ ನ್ಯಾಯಾಲಯದ ಆದೇಶದ ಜಾರಿಗಾಗಿ ಹಾವೇರಿ ಜಿಲ್ಲೆ, ಬ್ಯಾಡಗಿ ತಾಲ್ಲೂಕಿನ ಅಂಗಾರಗಟ್ಟಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮಾಸಣಗಿ ಮತ್ತು ಹಿರೇನಂದಿಹಳ್ಳಿ ಗ್ರಾಮಗಳ ಜಮೀನುಗಳಿಗೆ ಭೂಬಾಡಿಗೆ ಅಥವಾ ಬೆಳೆ ನಷ್ಟ ಪರಿಹಾರ ಧನದ ಬಗ್ಗೆ ಹಾವೇರಿ ಉಪ ವಿಭಾಗಾಧಿಕಾರಿಗಳು ದಿನಾಂಕ 13/08/08ರಂದು ಹೊರಡಿಸಿದ ಐತೀರ್ಪಿನಂತೆ ರೂ.38,36,381–00ಗಳ (ಮೂವತ್ತೆಂಟು ಲಕ್ಷದ ಮೂವತ್ತಾರು ಸಾವಿರದ ಮುನ್ನೂರ ಎಂಭತ್ತೊಂದು ರೂ.ಗಳು ಮಾತ್ರ) ಭೂಮಾಲೀಕರಿಗೆ ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ.

ಈ ವೆಚ್ಚವನ್ನು 2008–09ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂ: ಎಫ್‌ಡಿ 21 ಟಿಎಫ್‌ಪಿ 2006 ದಿನಾಂಕ 02/09/2006ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 154

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ರೈತ ಕಾಯಕ ಕೆರೆ ಕಾರ್ಯಕ್ರಮದಡಿ ದಾವಣಗೆರೆ ಜಿಲ್ಲೆ, ಹೊನ್ನಾಳಿ ತಾಲ್ಲೂಕು, ಸವಳಂಗ ಹೊಸಕೆರೆ ಸಮಗ್ರ ಅಭಿವೃದ್ಧಿ ಕಾಮಗಾರಿಯ ಇ.ಐ.ಆರ್.ಎಲ್. ಗೆ ಅನುಮೋದನೆ ನೀಡುವ ಬಗ್ಗೆ.

**ಓದಲಾಗಿದೆ:**
1. ದಿನಾಂಕ 19/07/06ರ ಜಂಟಿ ನಿರ್ದೇಶಕರು, ಬೆಂಗಳೂರು ವಲಯ, ಕರ್ನಾಟಕ ಭೂಸೇನಾ ನಿಗಮ ನಿಯಮಿತ ರವರ ಪತ್ರದ ಸಂಖ್ಯೆ:ಜನಿ/ಕಭೂಸೇನಾ/ಬೆಂವ/ರೈಕಾಕೆ/2006–07/615.
2. ಸರ್ಕಾರದ ಆದೇಶ ಸಂಖ್ಯೆ: ಸನೀಇ 241 ಕೆಜಿದು 2000, ದಿನಾಂಕ 04/01/2003.
3. ಸರ್ಕಾರದ ಆದೇಶ ಸಂಖ್ಯೆ: ಸನೀಇ 241 ಕೆಜಿದು 2000(ಭಾಗ–2) ದಿನಾಂಕ 17/03/2003.
4. ದಿನಾಂಕ 03/10/08ರ ಪತ್ರ ವ್ಯವಹಾರದೊಂದಿಗೆ ಅಂತ್ಯಗೊಂಡಿರುವ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ರವರ ಪತ್ರದ ಸಂಖ್ಯೆ: ಮುಸದ/ತಾಂ–4/ಸ.ಇಂ–10/ದಾವಣಗೆರೆ/ ಹೊನ್ನಾಳಿ/ಸವಳಂಗ/ಇಐಆರ್‌ಎಲ್/2008–09/3762.

**ಪ್ರಸ್ತಾವನೆ:**

ಮೇಲೆ (1)ರಲ್ಲಿ ಓದಲಾದ ಪತ್ರದಲ್ಲಿ ಕರ್ನಾಟಕ ಭೂಸೇನಾ ನಿಗಮ ನಿಯಮಿತದ ಜಂಟಿ ನಿರ್ದೇಶಕರು ನಿಗಮದ ವತಿಯಿಂದ ರೈತ ಕಾಯಕ ಕೆರೆ ಯೋಜನೆಯಡಿ ಕೈಗೊಳ್ಳಲಾದ ದಾವಣಗೆರೆ ಜಿಲ್ಲೆ, ಹೊನ್ನಾಳಿ ತಾಲ್ಲೂಕು ಸವಳಂಗ ಹೊಸಕೆರೆ ಅಭಿವೃದ್ಧಿ ಕಾಮಗಾರಿಯಲ್ಲಿ ಕೆರೆಯಲ್ಲಿ ಎತ್ತಿದ ಹೂಳನ್ನು ಹೊರಗೆ ಸಾಗಿಸಲು ಮಾಡಲಾದ ಸಾಗಣಿ ವೆಚ್ಚವನ್ನು ಪಾವತಿಸುವಂತೆ ಕೋರಿರುತ್ತಾರೆ.

ರೈತ ಕಾಯಕ ಕೆರೆ ಯೋಜನೆಯಡಿ 50.00 ಲಕ್ಷ ರೂ.ಗಳ ಅಂದಾಜು ವೆಚ್ಚದಲ್ಲಿ ದಾವಣಗೆರೆ ಜಿಲ್ಲೆ, ಹೊನ್ನಾಳಿ ತಾ: ಸವಳಂಗ ಕೆರೆಯನ್ನು ಕರ್ನಾಟಕ ಭೂಸೇನಾ ನಿಗಮಕ್ಕೆ ವಹಿಸಿ ಸಮಗ್ರ ಅಭಿವೃದ್ಧಿಪಡಿಸಲು ಮೇಲೆ (2)ರಲ್ಲಿ ಓದಲಾದ ದಿನಾಂಕ 04/01/2003ರ ಆದೇಶದಲ್ಲಿ ಮಂಜೂರಾತಿ ನೀಡಲಾಗಿದೆ. ಈ ಆದೇಶದಲ್ಲಿ ಕೆರೆಯಂಗಳದಲ್ಲಿ ಎತ್ತುವ ಹೂಳನ್ನು "ರೈತರು ತಮ್ಮ ಸ್ವಂತ ಖರ್ಚಿನಲ್ಲಿ ಸಾಗಣೆ ಮಾಡತಕ್ಕದ್ದು, ಪ್ರತ್ಯೇಕವಾಗಿ ಸಾಗಣೆ ವೆಚ್ಚ ನೀಡಲಾಗುವುದಿಲ್ಲ" ಎಂಬ ಷರತ್ತನ್ನು

ವಿಧಿಸಲಾಗಿತ್ತು. ನಂತರ ಈ ಷರತ್ತವನ್ನು ಮೇಲೆ (3)ರಲ್ಲಿ ಓದಲಾದ ದಿನಾಂಕ 17/03/03ರ ತಿದ್ದುಪಡಿ ಆದೇಶದಲ್ಲಿ ಕೈಬಿಡಲಾಗಿದೆ.

ಸವಳಂಗ ಹೊಸಕೆರೆ ಅಭಿವೃದ್ಧಿ ಕಾಮಗಾರಿಯ ಅಂದಾಜಿನಲ್ಲಿ ಸದರಿ ಕೆರೆಯಂಗಳದ ಹೂಳೆತ್ತಲು 24.00 ಲಕ್ಷ ರೂ.ಗಳನ್ನು ನಿಗದಿಪಡಿಸಲಾಗಿತ್ತು. ಈ ಮೊತ್ತದಲ್ಲಿ ಪ್ರತಿ ಘನ ಮೀ. ಹೂಳಿಗೆ ರೂ.15/–ಗಳಂತೆ 1,59,486 ಘ.ನ.ಮೀ. ಹೂಳೆತ್ತಬೇಕಾಗಿತ್ತು. ಆದರೆ, ನಿಗಮವು 89,345 ಘನ ಮೀ. ಮಾತ್ರ ಹೂಳೆತ್ತಿದೆ. ಈ ಹೂಳನ್ನು ಸಾಗಿಸಲು ಒಂದು ಕಿ.ಮೀ. ಗೆ 12.65 ರೂ.ಗಳಂತೆ ಒಟ್ಟು 11,30,214–00 ರೂ.ಗಳಾಗುತ್ತಿದ್ದು, ಸಾಗಣೆ ವೆಚ್ಚ ಅಂದಾಜಿನಲ್ಲಿ ಸೇರಿಲ್ಲದೆ ಇದ್ದುದರಿಂದ, ಇದನ್ನು ಹೆಚ್ಚುವರಿ ಕಾರ್ಯವೆಂದು ಪರಿಗಣಿಸಿ ಈ ಮೊತ್ತಕ್ಕೆ ತಯಾರಿಸಿದ ಇ.ಐ.ಆರ್.ಎಲ್. ಗೆ ಸಣ್ಣ ನೀರಾವರಿ ದಕ್ಷಿಣ ವಲಯದ ಮುಖ್ಯ ಇಂಜಿನಿಯರ್‌ರವರು ಮೇಲೆ (3)ರಲ್ಲಿ ಓದಲಾದ ದಿನಾಂಕ 03/10/2008ರ ಪತ್ರದಲ್ಲಿ ಸರ್ಕಾರದ ಅನುಮೋದನೆ ಕೋರಿ ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಕಾಮಗಾರಿಯಲ್ಲಿ ಉಂಟಾಗಿರುವ ಈ ಹೆಚ್ಚುವರಿ ವೆಚ್ಚವನ್ನು ಮಂಜೂರಾದ ಮೂಲ ಅಂದಾಜು ಮೊತ್ತ 50.00 ಲಕ್ಷ ರೂ.ಗಳಿಗೆ ಹೋಲಿಸಿದಾಗ ಶೇ.22.60ರಷ್ಟು ಹೆಚ್ಚುವರಿಯಾಗಿರುತ್ತದೆ.

ಪ್ರಸ್ತಾವನೆಯನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ನೀಡಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 94 ಆವಿಸಂ 2006 ಬೆಂಗಳೂರು, ದಿನಾಂಕ 02ನೇ ಜನವರಿ 2009**.

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ರೈತ ಕಾಯಕ ಕೆರೆ ಯೋಜನೆಯಡಿ ಕೈಗೊಳ್ಳಲಾದ ದಾವಣಗೆರೆ ಜಿಲ್ಲೆ, ಹೊನ್ನಾಳಿ ತಾಲ್ಲೂಕು ಸವಳಂಗ ಹೊಸಕೆರೆ ಅಭಿವೃದ್ಧಿ ಕಾಮಗಾರಿಯಲ್ಲಿ ಕರ್ನಾಟಕ ಭೂಸೇನಾ ನಿಗಮವು ನಿರ್ವಹಿಸಿದ ಹೂಳು ಸಾಗಿಸುವ ಸಾಗಣೆ ವೆಚ್ಚ 11.30 ಲಕ್ಷ ರೂ.ಗಳ (ಹನ್ನೊಂದು ಲಕ್ಷದ ಮೂವತ್ತು ಸಾವಿರ ರೂ.ಗಳು ಮಾತ್ರ) ವರ್ಕ್‌ಸ್ಲಿಪ್‌ಗೆ ಸರ್ಕಾರವು ಅನುಮೋದನೆ ನೀಡಿದೆ.

ಈ ವೆಚ್ಚವನ್ನು 2008–09ನೇ ಸಾಲಿನ ಆಯವ್ಯಯದ ಲೆಕ್ಕ ಶೀರ್ಷಿಕೆ "4702–00–101–1–06–139 ಹಳೆಯ ಮತ್ತು ಒಡೆದ ಕೆರೆಗಳ ಜೀರ್ಣೋದ್ಧಾರ ಮತ್ತು ಕೆರೆಯ ಹೂಳೆತ್ತುವುದು(ಯೋಜನೆ)" ಅಡಿಯಲ್ಲಿ ಭರಿಸತಕ್ಕದ್ದು.

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ: ಎಫ್‌ಡಿ 01 ಟಿಎಫ್‌ಪಿ 2002 ದಿನಾಂಕ 20/01/2003ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕ ಪ್ರತ್ಯಾಯೋಜನೆ ಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 269

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲ ಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ತುಮಕೂರು ಜಿಲ್ಲೆ, ಕೊರಟಗೆರೆ ತಾಲ್ಲೂಕು ಶ್ರೀನಿವಾಸಪುರ ಗ್ರಾಮದ ಕಾಟೇನಹಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು. ಇವರ ದಿನಾಂಕ 6/11/2008ರ ಪತ್ರ ಸಂಖ್ಯೆ:ಮುಸನೀ(ದ)/ಲೆಶಾ/ಲೆಸ–1/3/ಭೂಸ್ವಾಧೀನ/2008–09/2453.

**ಪ್ರಸ್ತಾವನೆ:**

ಮೇಲೆ ಓದಲಾದ ಬೆಂಗಳೂರು ಸಣ್ಣ ನೀರಾವರಿ ದಕ್ಷಿಣ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ತುಮಕೂರು ಜಿಲ್ಲೆ, ಕೊರಟಗೆರೆ ತಾಲ್ಲೂಕು ಶ್ರೀನಿವಾಸಪುರ ಗ್ರಾಮದ ಕಾಟೇನಹಳ್ಳಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಶ್ರೀನಿವಾಸಪುರ ಗ್ರಾಮದ ಜಮೀನುಗಳಿಗೆ ಮಧುಗಿರಿ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣ ಸಂಖ್ಯೆ:5/84ರಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 06/01/1977
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 20/02/1982

ಸದರಿ ಭೂಸ್ವಾಧೀನ ಪ್ರಕ್ರಿಯೆಯಲ್ಲಿ ಶ್ರೀನಿವಾಸಪುರ ಗ್ರಾಮದ ಸರ್ವೆ ನಂ. 23ರ 28 ಎಕರೆ ಸೇರಿತ್ತು. ಸದರಿ ಸರ್ವೆ ನಂ.ನ ಭೂ ಮಾಲಿಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಮಧುಗಿರಿಯ ಹಿರಿಯ ಶ್ರೇಣಿಯ ಸಿವಿಲ್ ನ್ಯಾಯಾಲಯದಲ್ಲಿ ದಾಖಲಿಸಿದ್ದ ಎಲ್.ಐ.ಸಿ ಪ್ರಕರಣ ಸಂಖ್ಯೆ:5/1984ರಲ್ಲಿ ದಿನಾಂಕ: 18/04/2006ರಂದು ನೀಡಿದ ತೀರ್ಪಿನಲ್ಲಿ ಹೆಚ್ಚಿನ ಪರಿಹಾರ ಧನ ಪಾವತಿಸಲು ಆದೇಶಿಸಿದೆ ಅಲ್ಲದೆ ಸದರಿ ತೀರ್ಪಿನ ಸರ್ವೆ ನಂ: 23ರ ವಿಸ್ತೀರ್ಣಕ್ಕೆ ಸಂಬಂಧಿಸಿದಂತೆ ಮಾನ್ಯ ಅಪೆಕ್ಸ್ ಕೋರ್ಟ್‌ನ (ಸರ್ವೋಚ್ಚ ನ್ಯಾಯಾಲಯ) ನಿರ್ದೇಶನದಂತೆ ಸಂಬಂಧಪಟ್ಟ ಕಂದಾಯ ಅಧಿಕಾರಿಗಳು ನಡೆಸಿದ ಸರ್ವೆಯಿಂದ

ಈ ಸರ್ವೆ ನಂ.ನಲ್ಲಿ ಒಟ್ಟು 39 ಎಕರೆ 11 ಗುಂಟೆ ಜಮೀನು ಬಂದಿದ್ದು ಈ ಜಮೀನು ಸಣ್ಣ ನೀರಾವರಿ ಕೆರೆಯಲ್ಲಿ ಮುಳುಗಡೆಯಾಗಿರುವುದರಿಂದ ಈ ಎಲ್ಲಾ ಕ್ಷೇತ್ರಕ್ಕೂ ಪರಿಹಾರ ಧನ ನೀಡುವಂತೆ ಮಾನ್ಯ ನ್ಯಾಯಾಲಯವು ಆದೇಶಿಸಿದೆ. ಈ ಬಗ್ಗೆ ಸಲ್ಲಿಸಿರುವ ಮುಟೇಷನ್ ಮತ್ತು ಆರ್.ಟಿ.ಸಿ ಪ್ರತಿಗಳಲ್ಲಿ ಸರ್ವೆ ನಂ: 23, ಹೊಸ ಸರ್ವೆ ನಂ: 29ರ 39 ಎಕರೆ 11 ಗುಂಟೆ ಜಮೀನು ಸರ್ಕಾರಿ ಕೆರೆಗೆ ಮುಳುಗಡೆ ಎಂಬುದಾಗಿ ನಮೂದಿಸಲಾಗಿದೆ. ಅದ್ದರಿಂದ ಈ ಒಟ್ಟು ವಿಸ್ತೀರ್ಣಕ್ಕೆ ಮಾನ್ಯ ನ್ಯಾಯಾಲಯವೂ ಹೆಚ್ಚಿನ ಪರಿಹಾರಕ್ಕೆ ಸೂಚನೆ ನೀಡಿದೆ. ಇದಕ್ಕೆ ಭೂ ಸ್ವಾಧೀನ ಕಾಯಿದೆ 18(1)ರಡಿ ಅವಕಾಶವಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವೂ ದಿನಾಂಕ 22/12/2007ರ ಪತ್ರ ಸಂಖ್ಯೆ: ಆರ್‌ಡಿ199ಎಲ್ಎಸಿ(ಎಲ್‌ಸಿ)07ರಲ್ಲಿ ತೀರ್ಮಾನಿಸಿದೆ.

ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆ ತೀರ್ಮಾನ ಕೈಗೊಂಡಿದ್ದರೂ ಸಹ ಭೂ ಸ್ವಾಧೀನ ಅಧಿಕಾರಿಗಳು ಮಾನ್ಯ ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ತುಮಕೂರು ಜಿಲ್ಲಾ ನ್ಯಾಯಾಲಯದಲ್ಲಿ ಸಲ್ಲಿಸಿದ್ದ ರೆಗ್ಯೂಲರ್ ಅಪಿಲ್ ಸಂಖ್ಯೆ:212/2007ರಲ್ಲಿಯ ದಿನಾಂಕ 18/08/2007ರ ತೀರ್ಪು ಭೂ ಮಾಲಿಕರ ಪರವಾಗಿ ಆಗಿದೆ.

ಸಿವಿಲ್ ನ್ಯಾಯಾಲಯದ ಆದೇಶದಲ್ಲಿ ತಿಳಿಸಿರುವಂತೆ ಮಾನ್ಯ ಸರ್ವೋಚ್ಚ ನ್ಯಾಯಾಲಯದ ಪ್ರಕರಣ ಎಐಆರ್ 1996 ಎಸ್‌ಸಿರಲ್ಲಿ ನೀಡಿರುವ ರೂಲಿಂಗ್‌ನಲ್ಲಿ ಭೂಸ್ವಾಧೀನದ ತಿದ್ದುಪಡಿ ಕಾಯಿದೆಯಲ್ಲಿನ ಸವಲತ್ತುಗಳು ದಿನಾಂಕ 30/04/1982ರಿಂದ 24/09/1984ರ ವರೆಗೆ ಯಾವ ಪ್ರಕರಣಗಳು ಸಿವಿಲ್ ನ್ಯಾಯಾಲಯದಲ್ಲಿ ಅಥವಾ ಭೂ ಸ್ವಾಧೀನ ಅಧಿಕಾರಿಗಳ ಮುಂದೆ ಬಾಕಿ ಇದ್ದಲ್ಲಿ ಅವುಗಳಿಗೂ ಅನ್ವಯವಾಗತಕ್ಕದ್ದು ಎಂಬುದಾಗಿ ತೀರ್ಪು ನೀಡಿದೆ. ಸದರಿ ಪ್ರಕರಣದಲ್ಲಿ ಪಾವತಿಸಬೇಕಾದ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್ಎಸಿ ಸಂಖ್ಯೆ | ಶ್ರೀನಿವಾಸಪುರ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 5/84 | 23 | | 59,14,332–00 |

* ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 132 ಭೂಸ್ವಾಪ್ರ 2008, ಬೆಂಗಳೂರು, ದಿನಾಂಕ: 2ನೇ ಜನವರಿ 2009**

ತುಮಕೂರು ಜಿಲ್ಲೆ, ಕೊರಟಗೆರೆ ತಾಲ್ಲೂಕು ಶ್ರೀನಿವಾಸಪುರ ಗ್ರಾಮದ ಕಾಟೇನಹಳ್ಳಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಶ್ರೀನಿವಾಸಪುರ ಗ್ರಾಮಕ್ಕೆ ಸೇರಿದ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.59,14,332–00ಗಳನ್ನು (ಐವತ್ತೊಂಭತ್ತು ಲಕ್ಷದ ಹದಿನಾಲ್ಕು ಸಾವಿರದ ಮುನ್ನೂರ ಮೂವತ್ತೆರಡು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2008–09ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂ:ಎಫ್‌ಡಿ 21 ಟಿಎಫ್‌ಪಿ 2006 ದಿನಾಂಕ 02/09/2006ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 270

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ಕೋಲಾರ ಜಿಲ್ಲೆ, ಬಂಗಾರಪೇಟೆ ತಾಲ್ಲೂಕು, ಕೊಪ್ಪ ದೊಡ್ಡಕೆರೆಯ ಪೋಷಕ ಕಾಲುವೆ ಅಭಿವೃದ್ಧಿ ಕಾಮಗಾರಿಯ ಟೆಂಡರ್ ಅಂಗೀಕರಿಸುವ ಕುರಿತು.

**ಓದಲಾಗಿದೆ:** ದಿನಾಂಕ 11/12/08ರ ಪತ್ರ ವ್ಯವಹಾರದೊಂದಿಗೆ ಅಂತ್ಯಗೊಂಡಿರುವ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ರವರ ಪತ್ರ ಸಂಖ್ಯೆ:ಮುಸದ/ತಾಂ–3/ಸ.ಇಂ.7/ ಕೋಲಾರ/ಬಂಗಾರಪೇಟೆ/ ಕೊಪ್ಪದೊಡ್ಡಕೆರೆ ಟೆಂಡರ್/2008/4380.

**ಪ್ರಸ್ತಾವನೆ:**

ಕೋಲಾರ ಜಿಲ್ಲೆ, ಬಂಗಾರಪೇಟೆ ತಾಲ್ಲೂಕು, ಕೊಪ್ಪ ದೊಡ್ಡಕೆರೆ ಪೋಷಕ ನಾಲೆ ಅಭಿವೃದ್ಧಿ ಕಾಮಗಾರಿಯ 49.95 ಲಕ್ಷ ರೂ.ಗಳ ಅಂದಾಜು ಪಟ್ಟಿಗೆ ಸರ್ಕಾರದ ಆದೇಶ ಸಂಖ್ಯೆ: ಸನೀಇ 42 ಕೆಜಿದು 2007, ದಿನಾಂಕ 07/03/07ರಲ್ಲಿ ಆಡಳಿತಾತ್ಮಕ ಅನುಮೋದನೆ ನೀಡಲಾಗಿದೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಕೋಲಾರ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಕರೆಯಲಾದ ಟೆಂಡರ್‌ನ ಪ್ರಕಟಣೆಯನ್ನು ದಿನಾಂಕ 08/01/07ರಂದು ಜಿಲ್ಲಾ ಟೆಂಡರ್ ಬುಲೆಟಿನ್‌ನಲ್ಲಿ ಹಾಗೂ ವಿಜಯ ಕರ್ನಾಟಕ ದಿನಪತ್ರಿಕೆಯಲ್ಲಿ ದಿನಾಂಕ 14/01/07ರಲ್ಲಿ ಪ್ರಕಟಿಸಲಾಗಿದೆ.

ಈ ಟೆಂಡರ್ ಕರೆಗೆ ಪ್ರತಿಕ್ರಯಿಸಿ ಖಾಲಿ ಟೆಂಡರ್ ಫಾರಂ ಪಡೆದ ಇಬ್ಬರು ಗುತ್ತಿಗೆದಾರರು ನಿಗದಿತ ದಿನದಂದು ಭರ್ತಿ ಮಾಡಿದ ಟೆಂಡರ್‌ಗಳನ್ನು ಸಲ್ಲಿಸಿರುತ್ತಾರೆ. ಸ್ವೀಕರಿಸಲಾದ ಟೆಂಡರ್‌ಗಳಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳ ವಿವರ ಕೆಳಕಂಡಂತಿದೆ:

| | |
|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | ರೂ.49,81,668/– |
| ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿದಾಗ ಟೆಂಡರಿಗೆ ಇಡಲಾದ ಮೊತ್ತ | ರೂ.60,25,836/– |

| ಕ್ರ. ಸಂ | ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ | ಪ್ರಸಕ್ತ ಸಾಲಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ |
|---|---|---|---|---|
| 1 | ವಿ.ನಾರಾಯಣಸ್ವಾಮಿ 1ನೇ ದರ್ಜೆ ಗುತ್ತಿಗೆದಾರರು, ಕೋಲಾರ | 75,60,127/– | 51.76 ಹೆಚ್ಚು | 25.46 ಹೆಚ್ಚು |
| 2 | ಎಸ್.ಕೃಷ್ಣನ್, 1ನೇ ದರ್ಜೆ ಗುತ್ತಿಗೆದಾರರು, ಕೋಲಾರ | 78,73,177/– | 58.04 ಹೆಚ್ಚು | 30.66 ಹೆಚ್ಚು |

ಮೇಲ್ಕಂಡಂತೆ ಶ್ರೀ ವಿ. ನಾರಾಯಣಸ್ವಾಮಿ, 1ನೇ ದರ್ಜೆ ಗುತ್ತಿಗೆದಾರರು ಇವರು ನಮೂದಿಸಿರುವ ಮೊತ್ತ ರೂ.75,60,127–00ಗಳು ಅತಿ ಕಡಿಮೆ ಮೊತ್ತವಾಗಿದ್ದು, ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಂತೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 25.46ರಷ್ಟು ಹೆಚ್ಚಾಗಿದ್ದು, ದರಗಳನ್ನು ಕಡಿಮೆ ಮಾಡಿಸುವ ಬಗ್ಗೆ ಮುಖ್ಯ ಇಂಜಿನಿಯರ್‌ರವರ ಮಟ್ಟದಲ್ಲಿ ಗುತ್ತಿಗೆದಾರರೊಂದಿಗೆ ಸಂಧಾನ ನಡೆಸಲಾಗಿದ್ದು, ಪ್ರಸಕ್ತ ಸಾಲಿನ ದರಗಳಂತೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತದ ಮೇಲೆ ಶೇ.18ರಷ್ಟು ಹೆಚ್ಚುವರಿ ಮೊತ್ತಕ್ಕೆ ಕಾಮಗಾರಿ ಕೈಗೊಳ್ಳಲು ಒಪ್ಪಿರುತ್ತಾರೆಂದು, ಆದರೆ ಚಾಲ್ತಿ ದರಪಟ್ಟಿಯ ಮೇಲೆ ಶೇ.6ಕ್ಕಿಂತ ಹೆಚ್ಚುವರಿ ದರವನ್ನು ಅಂಗೀಕರಿಸಲು ಮುಖ್ಯ ಇಂಜಿನಿಯರ್‌ರವರಿಗೆ ಅಧಿಕಾರ ಇಲ್ಲದೇ ಇದ್ದುದರಿಂದ, ಈ ವಿಷಯವನ್ನು ಇಲಾಖಾ ಟೆಂಡರ್ ಪರಿಶೀಲನಾ ಸಮಿತಿಯ ಮುಂದೆ ದಿನಾಂಕ 07/02/2008ರ ಸಭೆಯಲ್ಲಿ ಮಂಡಿಸಿದ್ದು, ಈ ಸಭೆಯಲ್ಲಿ ಗುತ್ತಿಗೆದಾರರ ಮನವಿಯನ್ನು ಕೂಲಂಕಷವಾಗಿ ಪರಿಶೀಲಿಸಿದ ನಂತರ ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿದಾಗ ಪರಿಷ್ಕರಿಸಿದ ಟೆಂಡರಿಗಿಡಲಾದ ಮೊತ್ತದ ಮೇಲೆ ಶೇಕಡ 12.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ.67,48,936–00ಗಳಿಗೆ ಕಾಮಗಾರಿಯನ್ನು ಶ್ರೀ ವಿ. ನಾರಾಯಣಸ್ವಾಮಿ, 1ನೇ ದರ್ಜೆ ಗುತ್ತಿಗೆದಾರರು, ಕೋಲಾರ ಇವರಿಗೆ ವಹಿಸಲು ತೀರ್ಮಾನಿಸಲಾಯಿತು. ಅದರಂತೆ ಶ್ರೀ ವಿ. ನಾರಾಯಣಸ್ವಾಮಿ, 1ನೇ ದರ್ಜೆ ಗುತ್ತಿಗೆದಾರರು ಇವರ ಟೆಂಡರ್‌ನ್ನು ಅಂಗೀಕರಿಸಲು ಮೇಲೆ ಓದಲಾದ ದಿನಾಂಕ 11/12/08ರ ಪತ್ರದಲ್ಲಿ ಮುಖ್ಯ ಇಂಜಿನಿಯರ್‌ರವರು ಸರ್ಕಾರದ ಅನುಮೋದನೆಯನ್ನು ಕೋರಿರುತ್ತಾರೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 02 ಕೆಜಿದು 2008, ಬೆಂಗಳೂರು, ದಿನಾಂಕ 12ನೇ ಜನವರಿ 2009.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಕೋಲಾರ ಜಿಲ್ಲೆ, ಬಂಗಾರಪೇಟೆ ತಾಲ್ಲೂಕು, ಕೊಪ್ಪ ದೊಡ್ಡಕೆರೆ ಪೋಷಕ ಕಾಲುವೆ ಅಭಿವೃದ್ಧಿ ಕಾಮಗಾರಿಯ ಮಂಜೂರಾದ ಅಂದಾಜು ಪಟ್ಟಿ ಹಾಗೂ ಪ್ರಸಕ್ತ ಸಾಲಿನ ದರಪಟ್ಟಿಯಂತೆ ಪರಿಷ್ಕರಿಸಿದ ಟೆಂಡರಿಗೆ ಇಡಲಾದ ಮೊತ್ತ ರೂ.60,23,836–00ಗಳ ಮೇಲೆ ಶೇಕಡ 12.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ.67,48,936–00ಗಳಿಗೆ (ಅರವತ್ತೇಳು ಲಕ್ಷದ ನಲವತ್ತೆಂಟು ಸಾವಿರದ ಒಂಭೈನೂರ ಮೂವತ್ತಾರು ರೂ.ಗಳು ಮಾತ್ರ) ಶ್ರೀ ವಿ.ನಾರಾಯಣಸ್ವಾಮಿ, 1ನೇ ದರ್ಜೆ ಗುತ್ತಿಗೆದಾರರು, ಕೋಲಾರ ಇವರಿಗೆ ಕಾಮಗಾರಿಯನ್ನು ಕೆಳಕಂಡ ಷರತ್ತುಗಳೊಂದಿಗೆ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.
3. ಅಸಹಜ ದರಗಳನ್ನು ಸಮನ್ವಯಪಡಿಸಿಕೊಳ್ಳುವುದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ:ಎಫ್‌ಡಿ 01 ಟಿಎಫ್‌ಪಿ 2002, ದಿನಾಂಕ:20/01/2003ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 369

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲ ಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ಬೀದರ್ ಜಿಲ್ಲೆ, ಔರಾದ್ ತಾಲ್ಲೂಕು ಗಣೇಶಪುರ (ಯು) ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ವಾಗನಗೇರಾ ಮತ್ತು ಗಣೇಶಪುರ ಗ್ರಾಮಗಳ ಸ.ನಂ.ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 20/09/2008ರ ಪತ್ರದ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ ಭೂಸ್ವಾಪ್ರ/2008-09/5145.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಬೀದರ್ ಜಿಲ್ಲೆ, ಔರಾದ್ ತಾಲ್ಲೂಕು ಗಣೇಶಪುರ(ಯು) ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ವಾಗನಗೇರಾ ಮತ್ತು ಗಣೇಶಪುರ ಗ್ರಾಮಗಳ ಸರ್ವೆ ನಂಬರ್‌ಗಳಿಗೆ ಸೇರಿದ ಜಮೀನುಗಳಿಗೆ ಬೀದರ್‌ನ ಪ್ರಿನ್ಸಿಪಲ್ ಸಿವಿಲ್ ನ್ಯಾಯಾಲಯ (ಹಿರಿಯ ಶ್ರೇಣಿ)ವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 04/03/1999.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 26/06/2002.

ಭೂಸ್ವಾಧೀನಕ್ಕೊಳಪಟ್ಟ ಸ.ನಂ.78/2, 77, 36/3, 76/2ಗಳ ಭೂಮಾಲೀಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಬೀದರ್‌ನ ಹಿರಿಯ ಶ್ರೇಣಿ ಸಿವಿಲ್ ನ್ಯಾಯಾಲಯದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಸಂಖ್ಯೆ:68/04, 58/04, 70/04, 72/04ಗಳಲ್ಲಿ ಮಾನ್ಯ ನ್ಯಾಯಾಲಯವು ಮುಖ್ಯ ಪ್ರಕರಣದ ಎಲ್.ಎ.ಸಿ. 68/04ರಲ್ಲಿ ಸಾಮಾನ್ಯ ತೀರ್ಪು ನೀಡಿದೆ. ತೀರ್ಪಿನಲ್ಲಿ ಪ್ರತಿ ಎಕರೆಗೆ ರೂ.99,000/-ಗಳ ಮೌಲ್ಯ ನಿಗದಿಪಡಿಸಿ ಇದರ ಮೇಲೆ ಶಾಸನಬದ್ಧ ಇತರೆ ಸವಲತ್ತುಗಳನ್ನು ನೀಡಲು ಆದೇಶಿಸಿದೆ. ಈ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶದ ಮುಖ್ಯಸ್ಥರ ಪತ್ರ ಸಂಖ್ಯೆ:ಆರ್‌ಡಿ 443 ಎಲ್‌ಸಿಜಿ 08, ದಿನಾಂಕ 06/12/08ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ. | ಎಲ್.ಎ.ಸಿ. ಸಂಖ್ಯೆ | ಸರ್ವೆ ನಂ. | ಗ್ರಾಮ | ವಿಸ್ತೀರ್ಣ ಎ - ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 70/04 | 78/2 | ವಾಗನಗೇರಾ | 2-16 | 1432739 |
| | | 77 | | 2-00 | |
| 2 | 68/04 | 36/3 | ಗಣೇಶಪುರ | 0-05 | 41692 |
| 3 | 72/04 | 77 | ವಾಗನಗೇರಾ | 1-17 | 464009 |
| 4 | 58/04 | 76/2 | ವಾಗನಗೇರಾ | 2-00 | 651243 |
| | | | | | 2589683 |

- ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಪರಿಶೀಲಿಸಿ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 138 ಭೂಸ್ವಾಪ್ರ 2008, ಬೆಂಗಳೂರು, ದಿನಾಂಕ 13ನೇ ಜನವರಿ 2009.**

ಬೀದರ್ ಜಿಲ್ಲೆ, ಔರಾದ್ ತಾಲ್ಲೂಕು ಗಣೇಶಪುರ(ಯು) ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ವಾಗನಗೇರಾ ಮತ್ತು ಗಣೇಶಪುರ ಗ್ರಾಮಗಳ ಸರ್ವೆ ನಂಬರ್‌ಗಳಿಗೆ ಸೇರಿದ ಜಮೀನುಗಳಿಗೆ

ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.25,89,683-00ಗಳನ್ನು (ಇಪ್ಪತ್ತೈದು ಲಕ್ಷದ ಎಂಭತ್ತೊಂಭತ್ತು ಸಾವಿರದ ಆರುನೂರ ಎಂಭತ್ಮೂರು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2008-09ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702-00-800-1-00-ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂ:ಎಫ್‌ಡಿ 21 ಟಿಎಫ್‌ಪಿ 2006 ದಿನಾಂಕ 02/09/2006ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 370

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ತುಮಕೂರು ಜಿಲ್ಲೆ, ಕೊರಟಗೆರೆ ತಾಲ್ಲೂಕು, ಗುಂಡನಪಾಳ್ಯ ಬಳಿ ಹುಲಿಕುಂಟೆ ಮತ್ತು ಗುಂಡನಪಾಳ್ಯದ ಮಧ್ಯೆ ಚೆಕ್ ಡ್ಯಾಂ ನಿರ್ಮಾಣ ಕಾಮಗಾರಿಯ ಟೆಂಡರ್ ಅಂಗೀಕರಿಸುವ ಕುರಿತು.

**ಓದಲಾಗಿದೆ:**
1. ದಿನಾಂಕ 23/10/08ರ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ರವರ ಪತ್ರ ಸಂಖ್ಯೆ: ಮುಸದ/ತಾಂ-3/ಸ.ಇಂ.9/ 2007/3937.
2. ಅಧ್ಯಕ್ಷರು, ಟೆಂಡರ್ ಪರಿಶೀಲನಾ ಸಮಿತಿ, ಸಣ್ಣ ನೀರಾವರಿ ಇಲಾಖೆ ಹಾಗೂ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ಇವರ ದಿನಾಂಕ 04/12/08ರ ಪತ್ರ ಸಂಖ್ಯೆ: ಮುಸದ/ ಆಪ್ತಶಾಖೆ/ಟೆಂಡರ್/08-09/4329

**ಪ್ರಸ್ತಾವನೆ:**

ತುಮಕೂರು ಜಿಲ್ಲೆ, ಕೊರಟಗೆರೆ ತಾಲ್ಲೂಕು, ಗುಂಡನಪಾಳ್ಯ ಬಳಿ ಹುಲಿಕುಂಟೆ ಮತ್ತು ಗುಂಡನಪಾಳ್ಯದ ಮಧ್ಯೆ ಚೆಕ್ ಡ್ಯಾಂ ನಿರ್ಮಾಣ ಕಾಮಗಾರಿಯ 48.50 ಲಕ್ಷ ರೂ.ಗಳ ಅಂದಾಜಿಗೆ ಸರ್ಕಾರದ ಆದೇಶ ಸಂಖ್ಯೆ:ಸನೀಇ 46 ಅಪಿಬಂ 2008, ದಿನಾಂಕ 25/03/2008ರಲ್ಲಿ ಆಡಳಿತಾತ್ಮಕ ಅನುಮೋದನೆ ನೀಡಿದೆ ಹಾಗೂ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ರವರು ಸಿಇಆರ್ ಸಂ;10/08-09, ದಿನಾಂಕ 16/06/08ರಲ್ಲಿ ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ತುಮಕೂರು ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ದ್ವಿಲಕೋಟೆ ಪದ್ಧತಿಯಲ್ಲಿ ಕರೆಯಲಾದ ಟೆಂಡರ್‌ನ ಪ್ರಕಟಣೆಯನ್ನು ಈ ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | | |
|---|---|---|
| 1 | ತುಮಕೂರು ಜಿಲ್ಲಾ ಟೆಂಡರ್ ಬುಲೆಟಿನ್ | ದಿ:20/06/2008 |
| 2 | ಪ್ರಜಾವಾಣಿ ದಿನಪತ್ರಿಕೆ | ದಿ:04/07/2008 |

ಕಾರಣಾಂತರಗಳಿಂದ ಈ ಅಧಿಸೂಚನೆಯನ್ನು ಮುಂದೂಡಿ, ಅಂತಿಮವಾಗಿ ದಿನಾಂಕ 15/07/08ರಂದು ಪ್ರಕಟಣೆಯನ್ನು ಹೊರಡಿಸಿ ಭರ್ತಿ ಮಾಡಿದ ಟೆಂಡರ್ ಸಲ್ಲಿಸುವ ದಿನಾಂಕ 30/07/08ಕ್ಕೆ ನಿಗದಿಪಡಿಸಲಾಗಿತ್ತು. ಈ ಟೆಂಡರ್ ಕರೆಗೆ ಪ್ರತಿಕ್ರಯಿಸಿ ಖಾಲಿ ಟೆಂಡರ್ ಫಾರಂ ಪಡೆದ 43 ಜನ ಗುತ್ತಿಗೆದಾರರ ಪೈಕಿ ನಿಗದಿತ ದಿನದಂದು ಇಬ್ಬರು ಗುತ್ತಿಗೆದಾರರು ಮಾತ್ರ ಸಲ್ಲಿಸಿದ್ದ ಭರ್ತಿ ಮಾಡಿದ ಟೆಂಡರ್‌ಗಳನ್ನು ದಿನಾಂಕ 30/07/08ರಂದು ತೆರೆಯಲಾಗಿದ್ದು, ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳ ವಿವರ ಕೆಳಕಂಡಂತಿದೆ:

| | | | | |
|---|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | | ರೂ.48,35,925/- |
| ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿದಾಗ ಟೆಂಡರಿಗೆ ಇಡಲಾದ ಮೊತ್ತ | | | | ರೂ.50,73,129/- |
| ಕ್ರ.ಸಂ | ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ | ಪ್ರಸಕ್ತ ಸಾಲಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ |
| 1 | ಎ.ಡಿ.ಬಲರಾಮಯ್ಯ, 1ನೇ ದರ್ಜೆ ಗುತ್ತಿಗೆದಾರರು | 58,45,058/- | 20.87 ಹೆಚ್ಚು | 15.22 ಹೆಚ್ಚು |

| | | | | |
|---|---|---|---|---|
| 2 | ಎನ್.ಮಲ್ಲಿಕಾರ್ಜುನಯ್ಯ, 1ನೇ ದರ್ಜೆ ಗುತ್ತಿಗೆದಾರರು | 61,93,063/– | 28.04 ಹೆಚ್ಚು | 22.08 ಹೆಚ್ಚು |

ಮೇಲ್ಕಂಡಂತೆ ಕ್ರ.ಸಂ.1ರಲ್ಲಿರುವ ಶ್ರೀ ಎ.ಡಿ. ಬಲರಾಮಯ್ಯ, 1ನೇ ದರ್ಜೆ ಗುತ್ತಿಗೆದಾರರು ನಮೂದಿಸಿರುವ ಮೊತ್ತ ರೂ.58,45,058–00ಗಳು ಅತಿ ಕಡಿಮೆ ಮೊತ್ತವಾಗಿದ್ದು, ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಂತೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 15.22ರಷ್ಟು ಹೆಚ್ಚಾಗಿದ್ದು, ಚಾಲ್ತಿ ದರಪಟ್ಟಿಯ ಮೇಲೆ ಶೇ.6ಕ್ಕಿಂತ ಹೆಚ್ಚುವರಿ ದರವನ್ನು ಅಂಗೀಕರಿಸಲು ಮುಖ್ಯ ಇಂಜಿನಿಯರ್‌ರವರಿಗೆ ಅಧಿಕಾರ ಇಲ್ಲದೇ ಇದ್ದುದರಿಂದ, ಸರ್ಕಾರದ ಅನುಮೋದನೆಗಾಗಿ ಮೇಲೆ (1)ರಲ್ಲಿ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ರವರು ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಈ ಪ್ರಕರಣವನ್ನು ಇಲಾಖಾ ಟೆಂಡರ್ ಪರಿಶೀಲನಾ ಸಮಿತಿಯ ಮುಂದೆ ಮಂಡಿಸುವಂತೆ ಸೂಚಿಸಿದ್ದರ ಮೇರೆಗೆ ಗುತ್ತಿಗೆದಾರರು ಸೂಚಿಸಿರುವ ದರಗಳನ್ನು ಕಡಿಮೆಗೊಳಿಸುವ ಸಲುವಾಗಿ ಗುತ್ತಿಗೆದಾರರೊಂದಿಗೆ ಸಂಧಾನ ನಡೆಸಲು ದಿನಾಂಕ 18/11/2008ರಂದು ಇಲಾಖಾ ಟೆಂಡರ್ ಪರಿಶೀಲನಾ ಸಮಿತಿಯ ಸಭೆಯನ್ನು ಕರೆಯಲಾಗಿತ್ತು. ಸಭೆಯಲ್ಲಿ ಗುತ್ತಿಗೆದಾರರ ಮನವಿಯನ್ನು ಕೂಲಂಕಷವಾಗಿ ಪರಿಶೀಲಿಸಿದ ನಂತರ ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿದಾಗ ಪರಿಷ್ಕರಿಸಿದ ಟೆಂಡರಿಗಿಡಲಾದ ಮೊತ್ತ ರೂ.50,73,129–00ಗಳ ಮೇಲೆ ಶೇಕಡ 12.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ.56,81,904–00ಗಳಿಗೆ ಕಾಮಗಾರಿಯನ್ನು ಶ್ರೀ ಎ.ಡಿ. ಬಲರಾಮಯ್ಯ, 1ನೇ ದರ್ಜೆ ಗುತ್ತಿಗೆದಾರರು, ಕೊರಟಗೆರೆ ಇವರಿಗೆ ವಹಿಸಲು ಸಭೆಯಲ್ಲಿ ತೀರ್ಮಾನಿಸಿದ್ದು, ಇದಕ್ಕೆ ಗುತ್ತಿಗೆದಾರರು ಸಮ್ಮತಿ ನೀಡಿರುವುದಾಗಿ ತಿಳಿಸಿ ಸಭೆಯ ನಡವಳಿಗಳೊಂದಿಗೆ ಸದರಿಯವರ ಟೆಂಡರ್‌ನ್ನು ಅಂಗೀಕರಿಸಲು ಮೇಲೆ (2)ರಲ್ಲಿ ಓದಲಾದ ಪತ್ರದಲ್ಲಿ ಅಧ್ಯಕ್ಷರು, ಟೆಂಡರ್ ಪರಿಶೀಲನಾ ಸಮಿತಿ, ಸಣ್ಣ ನೀರಾವರಿ ಇಲಾಖೆ ಹಾಗೂ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ಇವರು ಶಿಫಾರಸ್ಸು ಮಾಡಿರುತ್ತಾರೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 115 ಅಪಿಬಂ 2008, ಬೆಂಗಳೂರು, ದಿನಾಂಕ 12ನೇ ಜನವರಿ 2009.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ತುಮಕೂರು ಜಿಲ್ಲೆ, ಕೊರಟಗೆರೆ ತಾಲ್ಲೂಕು, ಗುಂಡನಪಾಳ್ಯ ಬಳಿ ಹುಲಿಕುಂಟೆ ಮತ್ತು ಗುಂಡನಪಾಳ್ಯದ ಮಧ್ಯೆ ಚೆಕ್ ಡ್ಯಾಂ ನಿರ್ಮಾಣ ಕಾಮಗಾರಿಯ ಮಂಜೂರಾದ ಅಂದಾಜು ಪಟ್ಟಿ ಹಾಗೂ ಪ್ರಸಕ್ತ ಸಾಲಿನ ದರಪಟ್ಟಿಯಂತೆ ಪರಿಷ್ಕರಿಸಿದ ಟೆಂಡರಿಗೆ ಇಡಲಾದ ಮೊತ್ತ ರೂ. 50,73,129–00ಗಳ ಮೇಲೆ ಶೇಕಡ 12.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 56,81,904–00ಗಳಿಗೆ (ಐವತ್ತಾರು ಲಕ್ಷದ ಎಂಭತ್ತೊಂದು ಸಾವಿರದ ಒಂಭೈನೂರ ನಾಲ್ಕು ರೂ.ಗಳು ಮಾತ್ರ) ಶ್ರೀ ಎ.ಡಿ. ಬಲರಾಮಯ್ಯ, 1ನೇ ದರ್ಜೆ ಗುತ್ತಿಗೆದಾರರು, ಕೊರಟಗೆರೆ ಇವರಿಗೆ ಕಾಮಗಾರಿಯನ್ನು ಕೆಳಕಂಡ ಷರತ್ತುಗಳೊಂದಿಗೆ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.
3. ಅಸಹಜ ದರಗಳನ್ನು ಸಮನ್ವಯಪಡಿಸಿಕೊಳ್ಳುವುದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ:ಎಫ್‌ಡಿ 01 ಟಿಎಫ್‌ಪಿ 2002, ದಿನಾಂಕ: 20/01/2003ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್.371

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲ ಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ಹಾವೇರಿ ಜಿಲ್ಲೆ, ರಾಣೆಬೆನ್ನೂರು ತಾಲ್ಲೂಕು ಕುದರಿಹಾಳ, ಹರಣಗಿರಿ ಏತ ನೀರಾವರಿ ಯೋಜನೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 13/11/2008ರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ 2008–09 6004.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಹಾವೇರಿ ಜಿಲ್ಲೆ, ರಾಣೆಬೆನ್ನೂರು ತಾಲ್ಲೂಕು ಕುದರಿಹಾಳ, ಹರಣಗಿರಿ ಏತ ನೀರಾವರಿ ಯೋಜನೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಕುದರಿಹಾಳ ಗ್ರಾಮದ ಜಮೀನುಗಳಿಗೆ ರಾಣೆಬೆನ್ನೂರು ಸಿವಿಲ್ ನ್ಯಾಯಾಲಯ (ಹಿರಿಯ ಶ್ರೇಣಿ) ಮತ್ತು ಪ್ರಿನ್ಸಿಪಲ್

ಜೆ.ಎಂ.ಎಫ್.ಸಿ. ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 15/12/88
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 23/05/90

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ರಾಣೆಬೆನ್ನೂರು ಸಿವಿಲ್ ನ್ಯಾಯಾಲಯ (ಹಿರಿಯ ಶ್ರೇಣಿ) ಮತ್ತು ಪ್ರಿನ್ಸಿಪಲ್ ಜೆ.ಎಂ.ಎಫ್.ಸಿ. ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣವನ್ನು ದಾಖಲಿಸಿದ್ದು, ಈ ಪ್ರಕರಣದಲ್ಲಿ ಮಾನ್ಯ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ.

ಈ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯು ಪತ್ರ ಸಂಖ್ಯೆ:ಆರ್‌ಡಿ 10 ಎಲ್ಎಸಿ(ಎಲ್‌ಸಿ) 2008, ದಿನಾಂಕ 31/01/08ರಲ್ಲಿ ಅಭಿಪ್ರಾಯ ನೀಡಿದೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣದ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್‌ಎಸಿ ಸಂಖ್ಯೆ | ಇ.ಪಿ. ಸಂಖ್ಯೆ | ಕುದರಿಹಾಳ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 1/95 | 123/07 | 131/1+2/ಂ+ಃ/1 | 0–34 | 5,72,182–00 |

- ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 38 ಭೂಸ್ವಾಪ್ರ 2008, ಬೆಂಗಳೂರು, ದಿನಾಂಕ 06ನೇ ಜನವರಿ 2009.**

ಹಾವೇರಿ ಜಿಲ್ಲೆ, ರಾಣೆಬೆನ್ನೂರು ತಾಲ್ಲೂಕು ಕುದರಿಹಾಳ, ಹರಣಗಿರಿ ಏತ ನೀರಾವರಿ ಯೋಜನೆಗಾಗಿ ಸ್ವಾಧೀನಪಡಿಸಿಕೊಂಡ ಕುದರಿಹಾಳ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.5,72,182–00ಗಳನ್ನು (ಐದು ಲಕ್ಷದ ಎಪ್ಪತ್ತೆರಡು ಸಾವಿರದ ನೂರ ಎಂಭತ್ತೆರಡು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2008–09ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂ: ಎಫ್‌ಡಿ 21 ಟಿಎಫ್‌ಪಿ 2006 ದಿನಾಂಕ 02/09/2006ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್.373 **ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ದಾವಣಗೆರೆ ಜಿಲ್ಲೆ ಹರಪನಹಳ್ಳಿ ತಾಲ್ಲೂಕು ತುಂಗಭದ್ರಾ ನದಿಗೆ ಅಡ್ಡಲಾಗಿ ಗರ್ಭಗುಡಿ ಹತ್ತಿರ ಸೇತುವೆ ಸಹಿತ ಬಾಂದಾರ ನಿರ್ಮಾಣ ಕಾಮಗಾರಿಯನ್ನು ಜಲಸಂಪನ್ಮೂಲ ಇಲಾಖೆಗೆ ವರ್ಗಾಯಿಸುವ ಬಗ್ಗೆ.

**ಓದಲಾಗಿದೆ:** 1. ಸರ್ಕಾರದ ಆದೇಶ ಸಂಖ್ಯೆ:ಸನೀಇ 53 ಸನೀಗು 98, ದಿನಾಂಕ 14/08/98,

2. ದಿನಾಂಕ 08/10/07ರ ಪತ್ರ ವ್ಯವಹಾರದೊಂದಿಗೆ ಅಂತ್ಯಗೊಂಡಿರುವ ಸಣ್ಣ ನೀರಾವರಿ ದಕ್ಷಿಣ ವಲಯದ ಮುಖ್ಯ ಇಂಜಿನಿಯರ್‌ರವರ ಪತ್ರ ಸಂಖ್ಯೆ: ಮುಇಂ/ ಸನೀ(ದ)/ತಾಂ–4/ ದಾವಣಗೆರೆ/ ಗರ್ಭಗುಡಿ/ 2007–08/6319.

**ಪ್ರಸ್ತಾವನೆ:**

ದಾವಣಗೆರೆ ಜಿಲ್ಲೆಯ (ಹಿಂದೆ ಬಳ್ಳಾರಿ ಜಿಲ್ಲೆಯ ವ್ಯಾಪ್ತಿಯಲ್ಲಿದ್ದ) ಹರಪನಹಳ್ಳಿ ಹಾಗೂ ದಾವಣಗೆರೆ ತಾಲ್ಲೂಕಿನ ಒಟ್ಟು 1520 ಹೆಕ್ಟೇರು ಜಮೀನುಗಳಿಗೆ ನೀರಾವರಿ ಸೌಲಭ್ಯ ಕಲ್ಪಿಸುವ ಉದ್ದೇಶದಿಂದ ಹರಪನಹಳ್ಳಿ ತಾಲ್ಲೂಕಿನ ಗರ್ಭಗುಡಿ ಗ್ರಾಮದ ಬಳಿ ತುಂಗಭದ್ರಾ ನದಿಗೆ ಅಡ್ಡಲಾಗಿ ಸೇತುವೆ ಸಹಿತ ಬಾಂದಾರ ನಿರ್ಮಾಣ ಮಾಡಲು 830.00 ಲಕ್ಷ ರೂ.ಗಳ ಅಂದಾಜು ಪಟ್ಟಿಗೆ ಮೇಲೆ (1)ರಲ್ಲಿ ಓದಲಾದ ಸರ್ಕಾರದ ಆದೇಶದಲ್ಲಿ ಅನುಮೋದನೆ ನೀಡಲಾಗಿದೆ. ಈ ಕಾಮಗಾರಿಯನ್ನು ನಿರ್ಮಾಣಕ್ಕಾಗಿ ನಬಾರ್ಡ್ ಸಂಸ್ಥೆಯ ಆರ್.ಐ.ಡಿ.ಎಫ್–VI ರಡಿ ರೂ.736.20ಲಕ್ಷಗಳ ಸಾಲ ಸೌಲಭ್ಯವು ಮಂಜೂರಾಗಿತ್ತು. ಈ ಕಾಮಗಾರಿಯನ್ನು ಅನುಷ್ಠಾನಗೊಳಿಸಲು ಕರ್ನಾಟಕ ರಾಜ್ಯ ನಿರ್ಮಾಣ ನಿಗಮಕ್ಕೆ ಸರ್ಕಾರದ ಆದೇಶ ಸಂಖ್ಯೆ:ನೀಇ 53 ಸನೀಗು 91 ದಿನಾಂಕ 20.11.1998ರಂತೆ ವಹಿಸಲಾಗಿತ್ತು.

ಸದರಿ ನಿಗಮವು ಕಾಮಗಾರಿಯನ್ನು ಪ್ರಾರಂಭಿಸಿ ರೂ.177.90 ಲಕ್ಷಗಳಷ್ಟು ಕಾಮಗಾರಿಯಲ್ಲಿ ಪ್ರಗತಿ ಸಾಧಿಸಿ ನಂತರ ತಾಂತ್ರಿಕ ಕಾರಣಗಳಿಂದಾಗಿ ಕಾಮಗಾರಿಯನ್ನು ಮೇ 2000 ರಲ್ಲಿ ಸ್ಥಗಿತಗೊಳಿಸಿತ್ತು. ಆ ಭಾಗದಲ್ಲಿಯ ರೈತರು ಹಾಗೂ ಸಾರ್ವಜನಿಕರ ಹಿತದೃಷ್ಟಿಯಿಂದ ಕಾಮಗಾರಿಯನ್ನು ಕೈಗೊಳ್ಳುವುದು ಅತ್ಯಾವಶ್ಯಕವೆಂದು ಭಾವಿಸಿ ಕಾಮಗಾರಿಯನ್ನು ಮುಂದುವರೆಸುವ ಬಗ್ಗೆ ತಾಂತ್ರಿಕ ಮೌಲ್ಯ ನಿರ್ಣಯ ಸಮಿತಿಯ ಸಲಹೆ/ ಸೂಚನೆಗಳಂತೆ ಕ್ರಮ ಕೈಗೊಂಡು ಕಾಮಗಾರಿಯ ಪರಿಷ್ಕೃತ ಅಂದಾಜು ಪಟ್ಟಿಯನ್ನು 36.75 ಕೋಟಿ ರೂ.ಗಳಿಗೆ ತಯಾರಿಸಿದ್ದು, ಈ ಪರಿಷ್ಕೃತ ಅಂದಾಜು ಪಟ್ಟಿಗೆ ಆಡಳಿತಾತ್ಮಕ ಅನುಮೋದನೆ ನೀಡುವಂತೆ ಮೇಲೆ (2)ರಲ್ಲಿ ಓದಲಾದ ಪತ್ರದಲ್ಲಿ ಸಣ್ಣ ನೀರಾವರಿ ದಕ್ಷಿಣ ವಲಯದ ಮುಖ್ಯ ಇಂಜಿನಿಯರ್‌ರವರು ಕೋರಿರುತ್ತಾರೆ.

ವಿಷಯವನ್ನು ಕೂಲಂಕಷವಾಗಿ ಪರಿಶೀಲಿಸಿ ಪ್ರಸ್ತಾಪಿಸಿರುವ ಈ ಯೋಜನೆಯನ್ನು ಜಲಸಂಪನ್ಮೂಲ ಇಲಾಖೆಗೆ ವರ್ಗಾಯಿಸಲು ತೀರ್ಮಾನಿಸಿ ಸರ್ಕಾರವು ಕೆಳಕಂಡಂತಿದೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 02 ನಯೋಕಾ 2005, ಬೆಂಗಳೂರು, ದಿನಾಂಕ 12ನೇ ಜನವರಿ 2009**.

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ 36.75 ಕೋಟಿ ರೂ.ಗಳ ಪರಿಷ್ಕೃತ ಅಂದಾಜು ವೆಚ್ಚದೊಂದಿಗೆ ದಾವಣಗೆರೆ ಜಿಲ್ಲೆ ಹರಪನಹಳ್ಳಿ ತಾಲ್ಲೂಕಿನ ತುಂಗಭದ್ರಾ ನದಿಗೆ ಅಡ್ಡಲಾಗಿ ಗರ್ಭಗುಡಿ ಹತ್ತಿರ ಸೇತುವೆ ಸಹಿತ ಬಾಂದಾರ ನಿರ್ಮಾಣವನ್ನು **ಜಲಸಂಪನ್ಮೂಲ ಇಲಾಖೆಯಿಂದ** ಅನುಷ್ಠಾನಗೊಳಿಸುವ ಷರತ್ತಿಗೊಳಪಟ್ಟು ಸರ್ಕಾರವು ಯೋಜನೆಗೆ ತಾತ್ವಿಕ ಒಪ್ಪಿಗೆ ನೀಡಿದೆ.

2) This Order falls within the purview of the provision to Sub Rule(2) of Rule 17 of the Karnataka Government (Transaction of Business) Rules, 1977, and is issued accordingly.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 375

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲ ಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ರಾಯನಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ತಾವರಗೇರಿ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಐತೀರ್ಪಿನಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 13/11/2008ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಭೂಸ್ವಾ/2008–09/6016

**ಪ್ರಸ್ತಾವನೆ:**

ಮೇಲೆ ಓದಲಾದ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ದಿನಾಂಕ 13/11/2008ರ ಪತ್ರದಲ್ಲಿ ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ರಾಯನಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ತಾವರಗೇರಿ ಗ್ರಾಮದ ಜಮೀನುಗಳಿಗೆ ಕೊಪ್ಪಳದ ಉಪ ವಿಭಾಗಾಧಿಕಾರಿಗಳು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಪ್ರಕಾರ ಉಪ ವಿಭಾಗಾಧಿಕಾರಿಗಳು ಹಾಗೂ ಭೂಸ್ವಾಧೀನಾಧಿಕಾರಿಗಳು, ಕೊಪ್ಪಳ ಇವರ ಐತೀರ್ಪಿನಂತೆ ಪರಿಹಾರ ಧನ ಪಾವತಿಸಲು ರೂ.15,59,342–00ಗಳನ್ನು ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಈ ಕೆರೆಯ ಮೂಲ ಭೂಸ್ವಾಧೀನ ಪ್ರಕ್ರಿಯೆಯ ವಿವರಗಳ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 01/02/1996
- ಉಪ ವಿಭಾಗಾಧಿಕಾರಿಗಳ ಐತೀರ್ಪಿನ ದಿನಾಂಕ 23/02/2001

ಭೂಸ್ವಾಧೀನಾದಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದ ತಾವರಗೇರಿ ಗ್ರಾಮದ ಸ.ನಂ.ಗಳ ಜಮೀನಿನ ಭೂಮಾಲೀಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳದ ಸಿವಿಲ್ ನ್ಯಾಯಾಲಯದಲ್ಲಿ

ಎಲ್.ಎ.ಸಿ. ಪ್ರಕರಣ ಸಂಖ್ಯೆ:37/02 ರಿಂದ 49/02 ಹಾಗೂ 60/02ರವರೆಗೆ ದಾಖಲಿಸಿ, ಹೆಚ್ಚಿನ ಪರಿಹಾರ ಧನಕ್ಕಾಗಿ ಆದೇಶ ಪಡೆದುಕೊಂಡಿದ್ದಾರೆ. ಈ ಆದೇಶವನ್ನು ಉಲ್ಲೇಖಿಸಿ ಸದರಿ ಭೂಸ್ವಾಧೀನ ಪ್ರಕರಣದಲ್ಲಿ ಸೇರಿದ್ದ ತಾವರಗೇರಿ ಗ್ರಾಮದ ಜಮೀನಿನ ಭೂಮಾಲೀಕರು ಅವರ ಜಮೀನಿಗೂ ಭೂಸ್ವಾಧೀನ ಕಾಯ್ದೆ 28(ಎ)ರಡಿ ಹೆಚ್ಚಿನ ಪರಿಹಾರ ಧನಕ್ಕಾಗಿ ಭೂಸ್ವಾಧೀನಾಧಿಕಾರಿಗಳಿಗೆ ಅರ್ಜಿ ಸಲ್ಲಿಸಿದ್ದರ ಮೇರೆಗೆ ಭೂಸ್ವಾಧೀನಾಧಿಕಾರಿಗಳು ಈ ಬಗ್ಗೆ ಪರಿಶೀಲಿಸಿ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಹೆಚ್ಚಿನ ಪರಿಹಾರ ಧನಕ್ಕೆ ದಿನಾಂಕ 11/01/08ರಂದು ಐತೀರ್ಪು ನೀಡಿದ್ದಾರೆ. ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪಾವತಿಸಬೇಕಾದ ಪರಿಹಾರ ಧನದ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ. ಸಂ | ತಾವರಗೇರಿ ಸ.ನಂ. | ವಿಸ್ತೀರ್ಣ ಎ-ಗುಂ. | ಭೂ.ಸ್ವಾ. ಕಾಯ್ದೆ ಕಲಂ 28(ಎ)ರಡಿ ಐತೀರ್ಪಿನ ಸಂಖ್ಯೆ ಮತ್ತು ದಿನಾಂಕ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 229 | 0-07 | ಕಂ/ಭೂಸ್ವಾ/ಸಾ/36/00-01/28(ಎ) ದಿನಾಂಕ 11/01/08 | 79675 |
| 2 | 207/2,1 | 0-18 | -do- | 204878 |
| 3 | 207/1/2 | 0-28 | -do- | 318698 |
| 4 | 229/1/1 | 0-06 | -do- | 68292 |
| 5 | 229 | 1-14 | -do- | 614629 |
| 6 | 228/1 | 0-24 | -do- | 273170 |
| | | | **ಒಟ್ಟು** | **1559342** |

ವಿಷಯವನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 153 ಭೂಸ್ವಾಪ್ರ 2008, ಬೆಂಗಳೂರು, ದಿನಾಂಕ 09ನೇ ಜನವರಿ 2009.**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ರಾಯನಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ತಾವರಗೇರಿ ಗ್ರಾಮದ ಮೇಲ್ಕಂಡ ಜಮೀನುಗಳಿಗೆ ಕೊಪ್ಪಳದ ಉಪ ವಿಭಾಗಾಧಿಕಾರಿಗಳು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಪ್ರಕಾರ ಉಪ ವಿಭಾಗಾಧಿಕಾರಿಗಳು, ಇಂಡಿ ಇವರು ದಿನಾಂಕ 11/01/2008ರ ಐತೀರ್ಪಿನಂತೆ ಪರಿಹಾರ ಧನದ ಮೊತ್ತ ರೂ. 15,59,342-00ಗಳನ್ನು (ಹದಿನೈದು ಲಕ್ಷದ ಐವತ್ತೊಂಭತ್ತು ಸಾವಿರದ ಮುನ್ನೂರ ನಲವತ್ತೆರಡು ರೂ.ಗಳು ಮಾತ್ರ) ಪ್ರಸ್ತಾವನೆಯಲ್ಲಿ ತಿಳಿಸಿರುವ ಸ.ನಂ.ಗಳಿಗೆ ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2008-09ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702-00-800-1-00-ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂ:ಎಫ್‌ಡಿ 21 ಟಿಎಫ್‌ಪಿ 2006 ದಿನಾಂಕ 02/09/2006ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 376

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಪುರ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಐತೀರ್ಪಿನಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 02/11/2008ರ ಪತ್ರ ಸಂಖ್ಯೆ: ಮುಇಂ/ಸನೀ(ಉ)ವ/ಭೂಸ್ವಾ/2008-09/6388

ಪ್ರಸ್ತಾವನೆ:

ಮೇಲೆ ಓದಲಾದ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ದಿನಾಂಕ 02/11/2008ರ ಪತ್ರದಲ್ಲಿ ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಪುರ ಗ್ರಾಮದ ಜಮೀನುಗಳಿಗೆ ಕೊಪ್ಪಳದ ಉಪ ವಿಭಾಗಾಧಿಕಾರಿಗಳು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಪ್ರಕಾರ ಉಪ ವಿಭಾಗಾಧಿಕಾರಿಗಳು ಹಾಗೂ ಭೂಸ್ವಾಧೀನಾಧಿಕಾರಿಗಳು, ಕೊಪ್ಪಳ ಇವರ ಐತೀರ್ಪಿನಂತೆ ಪರಿಹಾರ ಧನ ಪಾವತಿಸಲು ರೂ.31,28,370–00ಗಳನ್ನು ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಈ ಕೆರೆಯ ಮೂಲ ಭೂಸ್ವಾಧೀನ ಪ್ರಕ್ರಿಯೆಯ ವಿವರಗಳ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 04/01/2001
- ಉಪ ವಿಭಾಗಾಧಿಕಾರಿಗಳ ಐತೀರ್ಪಿನ ದಿನಾಂಕ 21/04/2003

ಪುರ ಗ್ರಾಮದ ಸ.ನಂ.14(ಎ)ರ 9–23 ಎಕರೆ ಮತ್ತು 114(ಅ)ನ 1–08 ಎಕರೆ ಜಮೀನಿಗೆ ಇದೇ ಕೆರೆಗೆ ಸ್ವಾಧೀನವಾದ ಭೂಸ್ವಾಧೀನ ಪ್ರಕ್ರಿಯೆಯಲ್ಲಿ ಸೇರಿದ್ದ ಪುರ ಗ್ರಾಮದ ಇತರೆ ಕೆಲವು ಸ.ನಂ.ಗಳಿಗೆ ಕೊಪ್ಪಳದ ಸಿವಿಲ್ ನ್ಯಾಯಾಲಯವು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ದಾಖಲಿಸಿದ್ದ ಎಲ್.ಎ.ಸಿ. ಸಂಖ್ಯೆ:121/05 (ಮುಖ್ಯ ಪ್ರಕರಣ), 120/05, 119/05, 118/05 ಮತ್ತು 117/05ರಲ್ಲಿ ನೀಡಿದ ಸಾಮಾನ್ಯ ಆದೇಶವನ್ನು ಆಧರಿಸಿ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಿ ಹೆಚ್ಚಿನ ಪರಿಹಾರ ಧನಕ್ಕೆ ದಿನಾಂಕ 24/06/08ರಂದು ಐತೀರ್ಪು ನೀಡಿದ್ದಾರೆ. ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪಾವತಿಸಬೇಕಾದ ಪರಿಹಾರ ಧನದ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ. ಸಂ | ಪುರ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಭೂ.ಸ್ವಾ. ಕಾಯ್ದೆ ಕಲಂ 28(ಎ)ರಡಿ ಐತೀರ್ಪಿನ ಸಂಖ್ಯೆ ಮತ್ತು ದಿನಾಂಕ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 14(ಎ) | 9–23 | ಕಂ/ಭೂಸ್ವಾ/14/2000–01/28(ಎ)/ಅಪೀಲು ದಿನಾಂಕ 24/06/08 | 2779966 |
| 2 | 114(ಅ) | 1–08 | -do- | 348404 |
| | | | **ಒಟ್ಟು** | **3128370** |

ವಿಷಯವನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 158 ಭೂಸ್ವಾಪ್ರ 2008, ಬೆಂಗಳೂರು, ದಿನಾಂಕ 09ನೇ ಜನವರಿ 2009.**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಪುರ ಗ್ರಾಮದ ಜಮೀನುಗಳಿಗೆ ಕೊಪ್ಪಳದ ಉಪ ವಿಭಾಗಾಧಿಕಾರಿಗಳು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಪ್ರಕಾರ ಉಪ ವಿಭಾಗಾಧಿಕಾರಿಗಳು, ಕೊಪ್ಪಳ ಇವರ ದಿನಾಂಕ 24/06/2008ರ ಐತೀರ್ಪಿನಂತೆ ಪರಿಹಾರ ಧನದ ಮೊತ್ತ ರೂ.31,28,370–00ಗಳನ್ನು (ಮೂವತ್ತೊಂದು ಲಕ್ಷದ ಇಪ್ಪತ್ತೆಂಟು ಸಾವಿರದ ಮುನ್ನೂರ ಎಪ್ಪತ್ತು ರೂ.ಗಳು ಮಾತ್ರ) ಪ್ರಸ್ತಾವನೆಯಲ್ಲಿ ತಿಳಿಸಿರುವ ಸ.ನಂ.ಗಳಿಗೆ ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2008–09ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂ: ಎಫ್‌ಡಿ 21 ಟಿಎಫ್‌ಪಿ 2006 ದಿನಾಂಕ 02/09/2006ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 377

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ಜಲಸಂಪನ್ಮೂಲ ಸಚಿವಾಲಯ**

**ವಿಷಯ:** ಗುಲ್ಬರ್ಗಾಜಿಲ್ಲೆ, ಅಫಜಲಪುರ ತಾಲ್ಲೂಕು ದೇವಲಗಾಣಗಪುರ ಗ್ರಾಮದ ಹತ್ತಿರ ಬ್ರೀಜ್ ಕಂ–ಬ್ಯಾರೇಜ್ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಧನ ಪಾವತಿಸುವ ಕುರಿತು

**ಓದಲಾಗಿದೆ** ಮುಖ್ಯಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ :09/01/2009ರ ಪತ್ರ ಸಂಖ್ಯೆ:ಮುಇಂ/ಸನೀ/(ಉ)ವ/ಬಿಜಾ/ಭೂಸ್ವಾಪ್ರ/2008–09/146.

**ಪ್ರಸ್ತಾವನೆ:–**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಗುಲ್ಬರ್ಗಾ ಜಿಲ್ಲೆ, ಅಫಜಲಪುರ ತಾಲ್ಲೂಕು, ದೇವಲಗಾಣಗಪುರ ಗ್ರಾಮದ ಹತ್ತಿರ ಬ್ರೀಜ್ ಕಂ–ಬ್ಯಾರೇಜ್ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯವು ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರ ಧನ ಪಾವತಿಸಲು ರೂ. 83,032/–ಗಳ ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 05/06/2003.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ: 10/08/2004.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಗುಲ್ಬರ್ಗಾ ಸಿವಿಲ್ ನ್ಯಾಯಾಲಯದಲ್ಲಿ ಪ್ರಕರಣ ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ.

ಸಿವಿಲ್ ನ್ಯಾಯಾಲಯ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯ ಪತ್ರ ಸಂಖ್ಯೆ: ಲಾ 788 ಎಲ್‌ಎಸ್‌ಪಿ ದಿನಾಂಕ: 15/06/2007ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣದ ವಿವರ ಕೆಳಕಂಡಂತಿದೆ:

| ಕ್ರ. ಸಂ. | ಎಲ್‌ಎಸಿ ಪ್ರಕರಣ ಸಂಖ್ಯೆ | ಇಟಗಾ ಗ್ರಾಮದ ಸ.ನಂ | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 01 | 114/05 | 172/5 | 1–05 | 83,032/– |

- **ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.**

ಪ್ರಸ್ತಾವನೆಯನ್ನು ಕೂಲಂಕುಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 11 ಭೂಸ್ವಾಪ್ರ 2009 ಬೆಂಗಳೂರು, ದಿನಾಂಕ:06ನೇ ಫೆಬ್ರವರಿ 2009**

ಗುಲ್ಬರ್ಗಾ ಜಿಲ್ಲೆ, ಅಫಜಲಪುರ ತಾಲ್ಲೂಕು, ದೇವಲಗಾಣಗಪುರ ಗ್ರಾಮದ ಹತ್ತಿರ ಬ್ರೀಡ್ಜ್ ಕಂ ಬ್ಯಾರೇಜ್ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಇಟಗಾ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ನ ಜಮೀನಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕ ಹಾಕಿದ ಪರಿಹಾರ ಧನ ಮೊತ್ತ ರೂ. 83,032/–ಗಳನ್ನು (ಎಂಭತ್ತಮೂರು ಸಾವಿರದ ಮೂವತ್ತೆರಡು ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಡೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2008–09ನೇ ಸಾಲಿನ ಆಯವ್ಯಯದ ಲೆಕ್ಕ ಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳ ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 21 ಟಿಎಫ್‌ಪಿ 2006 ದಿನಾಂಕ: 02/09/2006ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ. ಸುಧಾಕರ ಶೆಟ್ಟಿ**

ಪಿ.ಆರ್. 662 ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ. (ಸಣ್ಣ ನೀರಾವರಿ).

**ವಿಷಯ:** ಚಿಕ್ಕಬಳ್ಳಾಪುರ ಜಿಲ್ಲೆ ಗೌರಿಬಿದನೂರು ತಾಲ್ಲೂಕಿನ ಗುಯ್ಯಲಹಳ್ಳಿ ಕೆರೆಯಲ್ಲಿ ಮೆ:ಪೆಗಾಸಸ್ ಸಂಸ್ಥೆ, ಬೆಂಗಳೂರು ರವರು ಬೋಟ್ ಶಿಪ್ ತರಬೇತಿ ನಡೆಸಲು ಅನುಮತಿ ಬಗ್ಗೆ.

**ಓದಲಾಗಿದೆ** ದಿನಾಂಕ:03/01/2009ರಂದು ಕೊನೆಗೊಂಡ ಮುಖ್ಯಇಂಜಿನಿಯರ್,ಸಣ್ಣನೀರಾವರಿ (ದಕ್ಷಿಣ) ವಲಯ, ಬೆಂಗಳೂರು ರವರ ಪತ್ರಸಂಖ್ಯೆ:ಮುಸದ/ತಾಂ.3/ಸ.ಇಂ.7/ಚಿ.ಪುರ/ಗೌರಿಬಿದನೂರು/ಗುಯ್ಯಲಹಳ್ಳಿ ಕೆರೆ/ ಪೆಗಾಸಸ್/2008/42

**ಪ್ರಸ್ತಾವನೆ:–**

ಮೆ: ಪೆಗಾಸಸ್ ಸಂಸ್ಥೆ, ಬೆಂಗಳೂರು ರವರು ಚಿಕ್ಕಬಳ್ಳಾಪುರ ಜಿಲ್ಲೆ ಗೌರಿಬಿದನೂರು ತಾಲ್ಲೂಕು ಗುಯ್ಯಲಹಳ್ಳಿ ಕೆರೆಯಲ್ಲಿ ವಿವಿಧ ಸಂಘ ಸಂಸ್ಥೆಯ ಅಭ್ಯರ್ಥಿಗಳಿಗೆ ತುರ್ತಿನ ಸಮಯದಲ್ಲಿ ನೀರಿನಿಂದ ಉಂಟಾಗಬಹುದಾದ ಆಕಸ್ಮಿಕಗಳಿಂದ ಪಾರು ಮಾಡಲು ದೋಣಿ ಮತ್ತು ತೆಪ್ಪಗಳನ್ನು ಬಳಸಿ ಅಪತ್ಕಾಲದಲ್ಲಿ ಪ್ರಾಣ ರಕ್ಷಣೆ ಮತ್ತು ಸಾರ್ವಜನಿಕ ಜೀವ ರಕ್ಷಣೆಗೆ ಸಂಬಂಧಿಸಿದಂತೆ ತರಬೇತಿ ನೀಡಲು ಉದ್ದೇಶಿಸಿದ್ದು, ಈ ತರಬೇತಿ ಕಾರ್ಯಕ್ರಮಕ್ಕಾಗಿ ಸದರಿ ಕೆರೆಯನ್ನು ಕೆಲವೊಂದು ಷರತ್ತುಗೊಳಪಟ್ಟು ಸಂಸ್ಥೆಗೆ ಬಳಸಿಕೊಳ್ಳಲು ಅನುಮತಿ ನೀಡಬಹುದೆಂದು ಮುಖ್ಯ ಇಂಜಿನಿಯರ್‌ರವರು ಮೇಲೆ ಓದಲಾದ ಪತ್ರದಲ್ಲಿ ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಪ್ರಸ್ತಾವನೆಯನ್ನು ಪರಿಶೀಲಿಸಲಾಗಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 92 ಮಸಾವಿ 2008 ಬೆಂಗಳೂರು, ದಿನಾಂಕ: 18ನೇ ಫೆಬ್ರವರಿ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಅಪತ್ಕಾಲದಲ್ಲಿ ನೀರಿನಿಂದ ಪ್ರಾಣ ರಕ್ಷಣೆ ಮತ್ತು ಸಾರ್ವಜನಿಕ ಜೀವ ರಕ್ಷಣೆಗೆ ಸಂಬಂಧಿಸಿದಂತೆ ತರಬೇತಿ ನೀಡುವ ಸಲುವಾಗಿ ಚಿಕ್ಕಬಳ್ಳಾಪುರ ಜಿಲ್ಲೆ ಗೌರಿಬಿದನೂರು ತಾಲ್ಲೂಕು ಗುಯ್ಯಲಹಳ್ಳಿ ಕೆರೆ ಅಂಗಳದ ಉತ್ತರ ಭಾಗದ ಸುಮಾರು 300x300 ಮೀಟರ್‌ಗಳಷ್ಟು ವಿಸ್ತೀರ್ಣದ ಸುತ್ತಳತೆ ಜಾಗವನ್ನು ಮೆ: ಪೆಗಾಸಸ್ ಸಂಸ್ಥೆ, ಬೆಂಗಳೂರು ಇವರು ವಾರ್ಷಿಕ ರೂ. 6,000/– (ಆರು ಸಾವಿರ ರೂಪಾಯಿಗಳು ಮಾತ್ರ)ಗಳ ಶುಲ್ಕ ಪಡೆದು ಕೆಳಕಂಡ ಷರತ್ತುಗೊಳಪಟ್ಟು ಬಳಸಿಕೊಳ್ಳಲು ಸರ್ಕಾರವು ಅನುಮೋದನೆ ನೀಡಿದೆ.

1) ಈ ಅನುಮತಿಯು ಈ ಆದೇಶ ಹೊರಡಿಸಿದ ದಿನಾಂಕದಿಂದ 2ವರ್ಷಗಳ ಅವಧಿಗೆ ಮರು ನವೀಕರಿಸುವ ಷರತ್ತಿಗೊಳಪಟ್ಟಿದೆ.
2) ಸಂಸ್ಥೆಯು ಸದರಿ ಕೆರೆ ಅಥವಾ ಕೆರೆಯ ಯಾವುದೇ ಭಾಗಕ್ಕೆ ಹಾನಿಯಾಗದಂತೆ ಮುಂಜಾಗರುಕತೆ ವಹಿಸುವುದು. ಹಾನಿ ಉಂಟಾದಲ್ಲಿ ಸಂಸ್ಥೆಯೇ ಭರಿಸತಕ್ಕದ್ದು.
3) ಸಂಸ್ಥೆಯು ಕೆರೆಯನ್ನು ತೆಪ್ಪ ಹಾಗೂ ದೋಣಿ ಮೂಲಕ ತರಬೇತಿ ಕಾರ್ಯಕ್ರಮಕ್ಕಾಗಿ ಮಾತ್ರ ಬಳಸತಕ್ಕದ್ದು, ಯಾವುದೇ ವಾಣಿಜ್ಯ ಚಟುವಟಿಕೆಗಳಿಗೆ ಬಳಸತಕ್ಕದ್ದಲ್ಲ.
4) ಸಂಸ್ಥೆಯು ಸದರಿ ತರಬೇತಿ ನಡೆಸುವ ಸಲುವಾಗಿ ಮುಂಜಾಗ್ರತಾ ಕ್ರಮಕ್ಕಾಗಿ ಕಂದಾಯ ಇಲಾಖೆ, ಪೋಲೀಸ್ ಇಲಾಖೆ, ಜಲಮಂಡಳಿ, ಅಗ್ನಿಶಾಮಕ ದಳ, ವಿದ್ಯುತ್ ಮಂಡಳಿ ಇತ್ಯಾದಿಗಳಿಂದ ಅವಶ್ಯಕ ಪರವಾನಗಿ ಪಡೆದು ಕೊಳ್ಳುವುದು.
5) ತರಬೇತಿ ಸಮಯದಲ್ಲಿ ಯಾವುದೇ ಪ್ರಾಣಹಾನಿ ಅಥವಾ ಸಾವು ನೋವು ಸಂಭವಿಸಿದಲ್ಲಿ ಅದರ ಪೂರ್ಣ ಜವಾಬ್ದಾರಿಯನ್ನು ಸದರಿ ಸಂಸ್ಥೆಯೇ ಹೊರತಕ್ಕದ್ದು.
6) ಸದರಿ ಕೆರೆಯನ್ನು ಮೀನುಗಾರಿಕೆ ಹಾಗೂ ಇತರ ಉದ್ದೇಶಗಳಿಗಾಗಿ ಸರ್ಕಾರದಿಂದ ಅನುಮತಿ ನೀಡಿದ್ದಲ್ಲಿ, ಸಂಸ್ಥೆಯು ಈ ಬಗ್ಗೆ ಆಡಚಣೆ ಮಾಡತಕ್ಕದ್ದಲ್ಲ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ. ಸುಧಾಕರ ಶೆಟ್ಟಿ**

ಪಿ.ಆರ್. 669 ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ. (ಸಣ್ಣ ನೀರಾವರಿ).

**ವಿಷಯ:** ಶಿವಮೊಗ್ಗ ಜಿಲ್ಲೆ, ಶಿಕಾರಿಪುರ ತಾಲ್ಲೂಕು ಹೊಸೂರು ಹೋಬಳಿ ಹುಲುಗಿನ ಕಟ್ಟೆ ಮುರುಗಣ್ಣನ ಕೆರೆ ಏರಿ ಮತ್ತು ಕೋಡಿ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನು ಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ಇವರ ದಿನಾಂಕ 10/11/2008ರ ಪತ್ರ ಸಂಖ್ಯೆ:ಮುಸನೀ(ದ)/ಲೆಶಾ/ಲೆಸ1/ ಭೂಸ್ವಾಧೀನ/3/08–09/2475.

**ಪ್ರಸ್ತಾವನೆ:–**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ದಕ್ಷಿಣ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಶಿವಮೊಗ್ಗ ಜಿಲ್ಲೆ, ಶಿಕಾರಿಪುರ ತಾಲ್ಲೂಕು ಹೊಸೂರು ಹೋಬಳಿ ಹುಲುಗಿನ ಕಟ್ಟೆ ಮುರುಗಣ್ಣನ ಕೆರೆ ಏರಿ ಮತ್ತು ಕೋಡಿ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸೊರಬ ಸಿವಿಲ್ ನ್ಯಾಯಾಲಯವು (ಹಿರಿಯ ಶ್ರೇಣಿ) ಎಲ್.ಎ.ಸಿ. ಪ್ರಕರಣಗಳಲ್ಲಿ

ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 12/08/2000
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 19/05/2003

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಸೊರಬ ಸಿವಿಲ್ ನ್ಯಾಯಾಲಯ(ಹಿರಿಯ ಶ್ರೇಣಿ)ದಲ್ಲಿ ಭೂಸ್ವಾಧೀನ ಪ್ರಕರಣಗಳನ್ನು ದಾಖಲಿಸಿದ್ದು, ಈ ಪ್ರಕರಣಗಳಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯು ಅಭಿಪ್ರಾಯ ನೀಡಿದೆ.

**ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:**

| ಕ್ರ. ಸಂ | ಎಲ್‌ಎಸಿ ಪ್ರಕರಣ ಸಂಖ್ಯೆ | ಹೊಸೂರು ಹಾಗೂ ಹುಲುಗಿನಕಟ್ಟೆ/ ಹೊಸೂರು ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 40/07 | 77 | 0–11 | 66468 |
| 2 | 41/07 | 113/3 | 0–08 | 44177 |
| 3 | 43/07 | 109/ಪಿ | 2–00 | 441773 |
| 4 | 44/07 | 111/1 | 3–30 | 828325 |
| 5 | 46/07 | 109/2 | 3–00 | 662660 |
| 6 | 47/07 | 109/ಪಿ | 2–00 | 441773 |
| 7 | 48/07 | 109/2 | 2–00 | 441773 |
| | | 109/3 | 2–00 | 441773 |
| 8 | 49/07 | 108 | 1–39 | 436252 |
| 9 | 51/07 | 96 | 0–16 | 88355 |
| 10 | 53/07 | 105 | 6–30 | 1490985 |
| 11 | 56/07 | 107/3 | 3–29 | 822803 |
| 12 | 50/07 | 109/1 | 2–00 | 442775 |
| 13 | 52/07 | 94 | 0–22 | 121488 |
| 14 | 55/07 | 95/3 | 0–26 | 143576 |
| 15 | 54/07 | 104 | 1–00 | 220887 |
| 16 | 45/07 | 112/ಪಿ | 0–20 | 110443 |
| 17 | 42/07 | 113/1 | 0–04 | 22089 |
| | ಒಟ್ಟು | | | **7268375** |

- **ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.**

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 89 ಭೂಸ್ವಾಪ್ರ 2008, ಬೆಂಗಳೂರು, ದಿನಾಂಕ 25ನೇ ಫೆಬ್ರವರಿ 2009.**

ಶಿವಮೊಗ್ಗ ಜಿಲ್ಲೆ, ಶಿಕಾರಿಪುರ ತಾಲ್ಲೂಕು ಹೊಸೂರು ಹೋಬಳಿ ಹುಲುಗಿನ ಕಟ್ಟೆ ಕೆರೆ ಮುರುಗಣ್ಣನ ಕೆರೆ ಏರಿ ಮತ್ತು ಕೋಡಿ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪುಗಳಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.72,68,375–00ಗಳನ್ನು (ಎಪ್ಪತ್ತೆರಡು ಲಕ್ಷದ ಅರವತ್ತೆಂಟು ಸಾವಿರದ ಮುನ್ನೂರ ಎಪ್ಪತ್ತೈದು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

